RNI No. **KARBIL/2001/47147**

# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೮<br>Volume 148 | ಬೆಂಗಳೂರು, ಗುರುವಾರ, ಜುಲೈ ೧೮, ೨೦೧೩ (ಆಷಾಢ ೨೭, ಶಕ ವರ್ಷ ೧೯೩೫)<br>Bangalore, Thursday, July 18, 2013 (Ashadha 27, Shaka Varsha 1935) | ಸಂಚಿಕೆ ೨೯<br>Issue 29 |
|---|---|---|

## ಭಾಗ ೩

## ಸರ್ಕಾರದ ಮತ್ತು ಖಾಸಗಿ ಜಾಹೀರಾತುಗಳು, ಲೋಕಸೇವಾ ಆಯೋಗದ ಜಾಹೀರಾತುಗಳು, ನೇಮಕಾತಿ ಸಮಿತಿಗಳ ಜಾಹೀರಾತುಗಳು

### ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರ ಕಛೇರಿ, ಚಿಕ್ಕಮಗಳೂರು

**ಅಧಿಸೂಚನೆ ಸಂಖ್ಯೆ: ADMN–01/2013, ದಿನಾಂಕ: 12–06–2013.**

**ವಿಷಯ:** ಶೀಘ್ರಲಿಪಿಗಾರರು, ಬೆರಳಚ್ಚುಗಾರರು, ಬೆರಳಚ್ಚು ನಕಲುಗಾರರು, ಆದೇಶಜಾರಿಕಾರರು ಮತ್ತು ಸೇವಕರ ಹುದ್ದೆಗಳನ್ನು ಭರ್ತಿ ಮಾಡುವ ಸಲುವಾಗಿ ಅರ್ಜಿಗಳನ್ನು ಆಹ್ವಾನಿಸುತ್ತಿರುವ ಬಗ್ಗೆ.

**ಉಲ್ಲೇಖ:**
1. ಮಾನ್ಯ ಉಚ್ಚ ನ್ಯಾಯಾಲಯದ ಪತ್ರ ಸಂಖ್ಯೆ: LCA-II 54/2011 ದಿನಾಂಕ: 01–10–2011.
2. ಮಾನ್ಯ ಉಚ್ಚ ನ್ಯಾಯಾಲಯದ ಪತ್ರ ಸಂಖ್ಯೆ: LCA-II 128/2012 ದಿ: 14–09–2012 ಮತ್ತು ದಿನಾಂಕ: 21–01–2013.
3. ಮಾನ್ಯ ಉಚ್ಚ ನ್ಯಾಯಾಲಯದ ಪತ್ರ ಸಂಖ್ಯೆ: LCA-II 08/2011 ದಿನಾಂಕ: 17–01–2013.
4. ಈ ಕಛೇರಿಯ ಆದೇಶ ದಿನಾಂಕ : 11–06–2013.

ಮೇಲ್ಕಂಡ ಉಲ್ಲೇಖಗಳ ಅನ್ವಯ ಗೌರವಾನ್ವಿತ ಉಚ್ಚ ನ್ಯಾಯಾಲಯದವರು, (4+5) ಒಟ್ಟು 9 ಶೀಘ್ರಲಿಪಿಗಾರರು, 6–ಬೆರಳಚ್ಚುಗಾರರು, 1–ಬೆರಳಚ್ಚು ನಕಲುಗಾರರು, 1–ಆದೇಶಜಾರಿಕಾರರು ಮತ್ತು 12–ಸೇವಕರ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಅನುಮತಿ ನೀಡಿರುತ್ತಾರೆ.

ಭರ್ತಿ ಮಾಡಿದ ಅರ್ಜಿಗಳನ್ನು ಸಲ್ಲಿಸಲು ಕೊನೆಯ **ದಿನಾಂಕಃ 19–07–2013ರ ಸಂಜೆ 5–00 ಗಂಟೆ.** ಅರ್ಜಿ ಸಲ್ಲಿಸಬೇಕಾದ ವಿಳಾಸ.– **ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಚಿಕ್ಕಮಗಳೂರು ಜಿಲ್ಲೆ, ಚಿಕ್ಕಮಗಳೂರು.**

ಮೇಲ್ಕಂಡ ಅಧಿಸೂಚನೆಯ ಅನ್ವಯ ಜಿಲ್ಲಾ ಮತ್ತು ಸತ್ರ ನ್ಯಾಯಾಲಯ, ಚಿಕ್ಕಮಗಳೂರು ಘಟಕದಲ್ಲಿ ಖಾಲಿ ಇರುವ ಶೀಘ್ರಲಿಪಿಗಾರರು, ಬೆರಳಚ್ಚು/ಬೆರಳಚ್ಚು ನಕಲುಗಾರರು, ಆದೇಶಜಾರಿಕಾರರು ಮತ್ತು ಸೇವಕರ ಹುದ್ದೆಗಳಿಗೆ ಅರ್ಹ ಅಭ್ಯರ್ಥಿಗಳಿಂದ ಅರ್ಜಿಗಳನ್ನು ಆಹ್ವಾನಿಸಲಾಗಿದೆ. ನಿಗದಿಪಡಿಸಿದ ಅರ್ಜಿ ನಮೂನೆಯ ಬೆರಳಚ್ಚು ಪ್ರತಿ/ಗಣಕೀಕೃತ ಪ್ರತಿಯಲ್ಲಿಯೇ ಅಭ್ಯರ್ಥಿಗಳು ತಮ್ಮ ಸ್ವಂತ ಕೈಬರಹದಿಂದ ಎಲ್ಲಾ ಅಂಕಣಗಳನ್ನು ಜಾಗರೂಕತೆಯಿಂದ ಭರ್ತಿ ಮಾಡಬೇಕು.

**ಹುದ್ದೆಗಳ ವರ್ಗೀಕರಣ**

| ಕ್ರಮ. ಸಂಖ್ಯೆ | ಹುದ್ದೆಯ ಹೆಸರು | ಹುದ್ದೆ ಸಂಖ್ಯೆ | ವರ್ಗೀಕರಣ | ಮೀಸಲಾತಿ | | | | | | | |
|---|---|---|---|---|---|---|---|---|---|---|---|
| | | | | ಸಾ.ಅ | ಪ.ಜಾ. | ಪ.ಪಂ. | ಪ್ರ.–1 | II–ಎ | II –ಬಿ | III–ಎ | III –ಬಿ |
| 1 | ಶೀಘ್ರಲಿಪಿಗಾರರು | 4+5=9 | ಇತರೆ | – | – | 1 | – | – | – | – | |
| | | | ಗ್ರಾ.ಅ. | – | 1 | – | – | 1 | – | – | – |
| | | | ಮ.ಅ. | 1 | – | 1 | 1 | – | 1 | – | – |
| | | | ಅಂಗವಿಕಲ | 1 | – | – | – | – | – | – | – |
| | | | ಮಾ.ಸೈ. | 1 | – | – | – | – | – | – | – |

| ಕ್ರಮ. ಸಂಖ್ಯೆ | ಹುದ್ದೆಯ ಹೆಸರು | ಹುದ್ದೆ ಸಂಖ್ಯೆ | ವರ್ಗೀಕರಣ | ಮೀಸಲಾತಿ | | | | | | | |
|---|---|---|---|---|---|---|---|---|---|---|---|
| | | | | ಸಾ.ಅ | ಪ.ಜಾ. | ಪ.ಪಂ. | ಪ್ರ.–1 | II–ಎ | II –ಬಿ | III–ಎ | III –ಬಿ |
| 2 | ಬೆರಳಚ್ಚುಗಾರರು | **6** | ಇತರೆ | 1 | – | – | – | – | – | – | 1 |
| | | | ಗ್ರಾ.ಅ. | – | 1 | – | – | – | – | – | – |
| | | | ಮ.ಅ. | – | – | – | – | – | – | – | – |
| | | | ಅಂಗವಿಕಲ | 1 | – | – | 1 | – | – | – | – |
| | | | ಮಾ.ಸೈ. | 1 | – | – | – | – | – | – | – |
| 3 | ಬೆರಳಚ್ಚು– ನಕಲುಗಾರರು | **1** | ಮ.ಅ. | – | – | 1 | – | – | – | – | – |
| 4 | ಆದೇಶ–ಜಾರಿಕಾರರು | **1** | ಮ.ಅ. | – | – | 1 | – | – | – | – | – |
| 5 | ಸೇವಕರು | **12** | ಇತರೆ | 1 | – | – | – | – | – | 1 | 1 |
| | | | ಗ್ರಾ.ಅ. | 1 | 1 | – | – | 1 | – | – | – |
| | | | ಮ.ಅ. | 2 | – | – | – | – | – | – | – |
| | | | ಅಂಗವಿಕಲ | – | 1 | – | – | 1 | – | – | – |
| | | | ಕ.ಮಾ.ಅ. | 1 | – | – | – | – | – | – | – |
| | | | ಮಾ.ಸೈ. | 1 | – | – | – | – | – | – | – |
| | **ಒಟ್ಟು** | **29** | | **12** | **4** | **4** | **2** | **3** | **1** | **1** | **2** |

«zÁºðv:

| **ಶೀಘ್ರಲಿಪಿಗಾರರು** | **ಬೆರಳಚ್ಚುಗಾರರು** |
|---|---|
| 1. ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>**2.** ಕರ್ನಾಟಕ ಪ್ರೌಢ ಶಿಕ್ಷಣ ಪರೀಕ್ಷಾ ಮಂಡಳಿಯವರು ನಡೆಸುವ ಕನ್ನಡ ಮತ್ತು ಆಂಗ್ಲ ಪ್ರೌಢದರ್ಜೆ (Senior Grade) ಶೀಘ್ರಲಿಪಿ ಹಾಗೂ ಕನ್ನಡ ಮತ್ತು ಆಂಗ್ಲ ಬೆರಳಚ್ಚು ಪ್ರೌಢದರ್ಜೆ ಪರೀಕ್ಷೆ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು. | 1. ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>**2.** ಕರ್ನಾಟಕ ಪ್ರೌಢ ಶಿಕ್ಷಣ ಪರೀಕ್ಷಾ ಮಂಡಳಿಯವರು ನಡೆಸುವ ಕನ್ನಡ ಮತ್ತು ಆಂಗ್ಲ ಬೆರಳಚ್ಚು ಪ್ರೌಢದರ್ಜೆ (Senior Grade) ಪರೀಕ್ಷೆ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು. |
| **ಬೆರಳಚ್ಚು ನಕಲುಗಾರರು** | |
| 1. ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>**2.** ಕರ್ನಾಟಕ ಪ್ರೌಢ ಶಿಕ್ಷಣ ಪರೀಕ್ಷಾ ಮಂಡಳಿಯವರು ನಡೆಸುವ ಕನ್ನಡ ಮತ್ತು ಆಂಗ್ಲ ಕಿರಿಯದರ್ಜೆ (Junior Grade) ಪರೀಕ್ಷೆ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು. | **(ಈ ಮೂರು ಹುದ್ದೆಗಳಿಗೆ ಕಂಪ್ಯೂಟರ್ ಜ್ಞಾನ ಅಪೇಕ್ಷಣೀಯ)** |
| **ಜಾರಿಕಾರರು** | **ಸೇವಕರು** |
| 1. ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>**2.** ವಾಹನ ಚಾಲನಾ ಪರವಾನಗಿಯನ್ನು ಹೊಂದಿರುವ ಅಭ್ಯರ್ಥಿಗಳಿಗೆ ಆದ್ಯತೆ ನೀಡಲಾಗುವುದು. | 1. 7ನೇ ತರಗತಿ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>2. ಕನ್ನಡ ಭಾಷೆಯನ್ನು ಓದಲು ಮತ್ತು ಬರೆಯಲು ಬಲ್ಲವರಾಗಿರಬೇಕು. |

**ಅರ್ಜಿಯಲ್ಲಿ ಮೀಸಲಾತಿಗೆ ಸಂಬಂಧಿಸಿದ ಅಂಕಣದಲ್ಲಿ ಉಪಯೋಗಿಸಿದ ಸಂಕ್ಷಿಪ್ತ ಪದಗಳ ಅರ್ಥವನ್ನು ಈ ಕೆಳಕಂಡಂತೆ ಅರ್ಥೈಸಿಕೊಳ್ಳಬೇಕು.**

| | | |
|---|---|---|
| ಸಾ.ಅ. – ಸಾಮಾನ್ಯ ಅಭ್ಯರ್ಥಿ | ಪ.ಜಾ. – ಪರಿಶಿಷ್ಟ ಜಾತಿ | ಮಾ.ಸೈ. – ಮಾಜಿ ಸೈನಿಕ |
| ಪ.ಪಂ. – ಪರಿಶಿಷ್ಟ ಪಂಗಡ | ಪ್ರ.1 – ಪ್ರವರ್ಗ 1 | ಕ.ಮಾ.ಅ. – ಕನ್ನಡ ಮಾಧ್ಯಮ ಅಭ್ಯರ್ಥಿ |
| ಮ.ಅ. – ಮಹಿಳಾ ಅಭ್ಯರ್ಥಿ | ಗ್ರಾ.ಅ. – ಗ್ರಾಮೀಣ ಅಭ್ಯರ್ಥಿ | |

**ವಯೋಮಿತಿ (ಅರ್ಜಿ ಸಲ್ಲಿಸಲು ಕೊನೆಯ ದಿನಾಂಕಕ್ಕೆ ಅನುಗುಣವಾಗಿ)**

**ಕನಿಷ್ಠ ವಯೋಮಿತಿ :** 18 ವರ್ಷ

**ಗರಿಷ್ಠ ವಯೋಮಿತಿ :** ಸಾಮಾನ್ಯ ವರ್ಗ – 35 ವರ್ಷ

2ಎ /2ಬಿ /3ಎ /3ಬಿ – 38 ವರ್ಷ

ಪ.ಜಾ/ಪ.ಪಂ/ಪ್ರವರ್ಗ – 40 ವರ್ಷ

ಸರ್ಕಾರಿ ಸೇವೆಯಲ್ಲಿರುವವರಿಗೆ, ವಿಧವೆಯರಿಗೆ, ಮಾಜಿ ಸೈನಿಕರಿಗೆ ಹಾಗೂ ಅಂಗವಿಕಲರಿಗೆ ನಿಯಮಾನುಸಾರ ವಯೋಮಿತಿಯಲ್ಲಿ ಸಡಿಲಿಕೆ ನೀಡಲಾಗುವುದು.

**ವೇತನ ಶ್ರೇಣಿ :**

ಶೀಘ್ರಲಿಪಿಗಾರರು : 14550–350–15600–400–17200–450–19000–500–21000–600–24400–700–26700 ಮತ್ತು ಇತರೆ ಭತ್ಯೆಗಳು.

ಬೆರಳಚ್ಚು/ಬೆರಳಚ್ಚು ನಕಲುಗಾರರು : 11600–200–12000–250–13000–300–14200–350–15600–400–17200–450–19000–500–21000 ಮತ್ತು ಇತರೆ ಭತ್ಯೆಗಳು.

ಆದೇಶಜಾರಿಕಾರರು : 10400–200–12000–250–13000–300–14200–350–15600–400–16400 ಮತ್ತು ಇತರೆ ಭತ್ಯೆಗಳು.

ಸೇವಕರು : 9600–200–12000–250–13000–300–14200–350–14550 ಮತ್ತು ಇತರೆ ಭತ್ಯೆಗಳು.

**ಆಯ್ಕೆ ವಿಧಾನ:**

ಕರ್ನಾಟಕ ಅಧೀನ ನ್ಯಾಯಾಲಯಗಳು (ಮಿನಿಸ್ಟ್ರಿಯಲ್ ಮತ್ತು ಇತರೆ ಹುದ್ದೆಗಳು) (ನೇಮಕಾತಿ) (ತಿದ್ದುಪಡಿ) ನಿಯಮಗಳು 2007 ರ ಅನ್ವಯ ನೇರ ನೇಮಕಾತಿಯ ಮೂಲಕ ಆಯ್ಕೆ ಮಾಡಲಾಗುವುದು.

**1. ಶೀಘ್ರಲಿಪಿಗಾರರು :**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳು ಮತ್ತು ನಿಮಿಷ 1ಕ್ಕೆ 120 ಪದಗಳ ದರದಲ್ಲಿ 5 ನಿಮಿಷಗಳ ಉಕ್ತಲೇಖನವನ್ನು ತೆಗೆದುಕೊಂಡು ಉಕ್ತಲೇಖನವನ್ನು 40 ನಿಮಿಷಗಳಲ್ಲಿ ಅನುಲಿಪಿ ಮಾಡುವ ಅರ್ಹತಾ ಪರೀಕ್ಷೆಯಲ್ಲಿ ಗಳಿಸುವ ಅಂಕಗಳು ಮತ್ತು ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು. 1 ಹುದ್ದೆಗೆ 5 ಅಭ್ಯರ್ಥಿಗಳಂತೆ ಅತಿ ಹೆಚ್ಚು ಅಂಕ ಪಡೆದ ಅಭ್ಯರ್ಥಿಗಳನ್ನು ಸಂದರ್ಶನಕ್ಕೆ ಕರೆಯಲಾಗುವುದು. (1:5 ರ ಅನುಪಾತದಲ್ಲಿ)

**ಟಿಪ್ಪಣಿ:** ಅರ್ಹತಾ ಪರೀಕ್ಷೆಯು ಗರಿಷ್ಠ 100 ಅಂಕಗಳನ್ನು ಒಳಗೊಂಡಿದ್ದು, ಅದರಲ್ಲಿ ತೇರ್ಗಡೆಯಾಗಲು ಕನಿಷ್ಠ 50 ಅಂಕಗಳನ್ನು ಪಡೆಯಬೇಕು. ಮತ್ತು ಸಂದರ್ಶನವು 10 ಅಂಕಗಳನ್ನು ಒಳಗೊಂಡಿರುತ್ತದೆ.

**2. ಬೆರಳಚ್ಚುಗಾರರು/ ಬೆರಳಚ್ಚು ನಕಲುಗಾರರು :**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳು ಮತ್ತು 15 ನಿಮಿಷಗಳ ಉಕ್ತಲೇಖನದಲ್ಲಿ ಕೊಡುವ ವಿಷಯವನ್ನು ಬೆರಳಚ್ಚು ಮಾಡುವ ಅರ್ಹತಾ ಪರೀಕ್ಷೆಯಲ್ಲಿ ಗಳಿಸುವ ಅಂಕಗಳು ಮತ್ತು ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು. 1 ಹುದ್ದೆಗೆ 5 ಅಭ್ಯರ್ಥಿಗಳಂತೆ ಅತಿ ಹೆಚ್ಚು ಅಂಕ ಪಡೆದ ಅಭ್ಯರ್ಥಿಗಳನ್ನು ಸಂದರ್ಶನಕ್ಕೆ ಕರೆಯಲಾಗುವುದು. (1:5 ರ ಅನುಪಾತದಲ್ಲಿ)

**ಟಿಪ್ಪಣಿ:** ಅರ್ಹತಾ ಪರೀಕ್ಷೆಯು ಗರಿಷ್ಠ 100 ಅಂಕಗಳನ್ನು ಒಳಗೊಂಡಿದ್ದು, ಅದರಲ್ಲಿ ತೇರ್ಗಡೆಯಾಗಲು ಕನಿಷ್ಠ 50 ಅಂಕಗಳನ್ನು ಪಡೆಯಬೇಕು. ಮತ್ತು ಸಂದರ್ಶನವು 10 ಅಂಕಗಳನ್ನು ಒಳಗೊಂಡಿರುತ್ತದೆ.

**3. ಆದೇಶಜಾರಿಕಾರರು:**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳ ಆಧಾರದ ಮೇಲೆ 1 ಹುದ್ದೆಗೆ 25 ಅಭ್ಯರ್ಥಿಗಳಂತೆ (1:25ರ ಅನುಪಾತದಲ್ಲಿ) ಅತಿ ಹೆಚ್ಚು ಅಂಕ ಪಡೆದ ಅಭ್ಯರ್ಥಿಗಳನ್ನು ಪ್ರಕಟಿಸಿರುವ ಹುದ್ದೆಗಳಿಗೆ ಅನುಗುಣವಾಗಿ ಸಂದರ್ಶನಕ್ಕೆ ಕರೆಯಲಾಗುವುದು. ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು.

**ಟಿಪ್ಪಣಿ:** ಸಂದರ್ಶನವು 10 ಅಂಕಗಳನ್ನು ಒಳಗೊಂಡಿರುತ್ತದೆ.

**4. ಸೇವಕರು:**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳ ಆಧಾರದ ಮೇಲೆ 1 ಹುದ್ದೆಗೆ 10 ಅಭ್ಯರ್ಥಿಗಳಂತೆ (1:10 ರ ಅನುಪಾತದಲ್ಲಿ) ಅತಿ ಹೆಚ್ಚು ಅಂಕ ಪಡೆದ ಅಭ್ಯರ್ಥಿಗಳನ್ನು ಪ್ರಕಟಿಸಿರುವ ಹುದ್ದೆಗಳಿಗೆ ಅನುಗುಣವಾಗಿ ಸಂದರ್ಶನಕ್ಕೆ ಕರೆಯಲಾಗುವುದು. ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು.

**ಟಿಪ್ಪಣಿ:** ಸಂದರ್ಶನವು 10 ಅಂಕಗಳನ್ನು ಒಳಗೊಂಡಿರುತ್ತದೆ.

**ಅಭ್ಯರ್ಥಿಗಳನ್ನು 2 ವರ್ಷಗಳ ಕಾಲ ಪರೀಕ್ಷಣಾ ಅವಧಿಯಲ್ಲಿಡಲಾಗುವುದು.**

**ಲಗತ್ತಿಸಬೇಕಾದ ದಾಖಲಾತಿಗಳು:**

ಅಭ್ಯರ್ಥಿಗಳು ಈ ಕೆಳಕಂಡ ಪ್ರಮಾಣಪತ್ರಗಳ ಒಂದೊಂದು ಫೋಟೋ ಪ್ರತಿಗಳನ್ನು (Xerox Copy) ಸ್ವಯಂ ದೃಢೀಕರಿಸಿ ಅರ್ಜಿಯೊಂದಿಗೆ ಲಗತ್ತಿಸಬೇಕು. ಕೊನೆಯ ದಿನಾಂಕದ ನಂತರ ಸಲ್ಲಿಸಲಾದ ಯಾವುದೇ ಅರ್ಜಿಗಳನ್ನು ಪರಿಗಣಿಸಲಾಗುವುದಿಲ್ಲ.

1. ಹುದ್ದೆಗಳಿಗೆ ನಿಗದಿಪಡಿಸಲಾದ ವಿದ್ಯಾರ್ಹತೆಯ ಅಂಕಪಟ್ಟಿಗಳು ಹಾಗೂ ಪ್ರಮಾಣಪತ್ರಗಳು.

2. ಜನ್ಮದಿನಾಂಕವನ್ನು ನಮೂದಿಸಿರುವ ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯ ಪ್ರಮಾಣ ಪತ್ರ, ವರ್ಗಾವಣೆ ಪ್ರಮಾಣಪತ್ರ, / ಜನನ ದಿನಾಂಕವನ್ನು ತೋರಿಸುವ ಸಂಚಿತ ದಾಖಲೆಯ ಉಧೃತ ಭಾಗ
3. ಸೈನಿಕ ಸೇವೆಯಿಂದ ಬಿಡುಗಡೆಯಾದ /ಮುಕ್ತಿಹೊಂದಿದ ಬಗ್ಗೆ ಪ್ರಮಾಣಪತ್ರ. (ಮಾಜಿಸೈನಿಕ ಮೀಸಲಾತಿ ಕೋರಿದ್ದಲ್ಲಿ)
4. ಪರಿಶಿಷ್ಠ ಜಾತಿ/ಪರಿಶಿಷ್ಟ ಪಂಗಡ ನಮೂನೆ –ಡಿ ಯಲ್ಲಿ, ಪ್ರವರ್ಗ–1 ರ ಅಭ್ಯರ್ಥಿಗಳು ನಮೂನೆ–ಇ ಯಲ್ಲಿ ಮತ್ತು 2–ಎ, 2–ಬಿ, 3–ಎ, 3–ಬಿ ಅಭ್ಯರ್ಥಿಗಳು ನಮೂನೆ ಎಫ್ ರಲ್ಲಿ ಸಂಬಂಧಿಸಿದ ತಹಸೀಲ್ದಾರರಿಂದ ಜಾತಿ ಮತ್ತು ಆದಾಯ ಪ್ರಮಾಣಪತ್ರಗಳನ್ನು ಪಡೆದು ಲಗತ್ತಿಸಬೇಕು.
5. ಶಾಲಾ ಮುಖ್ಯೋಪಾಧ್ಯಾಯರು/ ಪ್ರಾಂಶುಪಾಲರಿಂದ ಪಡೆದ ಒಂದು ನಡತೆ ಪ್ರಮಾಣ ಪತ್ರ ಹಾಗೂ ಸ್ಥಳೀಯ ಗಣ್ಯ ವ್ಯಕ್ತಿಗಳಿಂದ ಪಡೆದ ಎರಡು ನಡತೆ ಪ್ರಮಾಣ ಪತ್ರಗಳು.
6. ಗ್ರಾಮೀಣ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ಸರ್ಕಾರಿ ಆದೇಶ ಸಂಖ್ಯೆ:ಸಿಆಸುಇ/96/ಸೇನನಿ/2005ದ ದಿನಾಂಕ: 10.08.2005 ರ ಪ್ರಕಾರ ನಿಗದಿತ ನಮೂನೆ–2 ರಲ್ಲಿ ಅಧಿಕೃತ ಅಧಿಕಾರಿಗಳಿಂದ ಪಡೆದು ಅದನ್ನು ಸಂಬಂಧಿಸಿದ ಕ್ಷೇತ್ರ ಶಿಕ್ಷಣಾಧಿಕಾರಿಗಳಿಂದ ಮೇಲು ಸಹಿ ಮಾಡಿಸಿ ಸಲ್ಲಿಸಬೇಕು. ಗ್ರಾಮೀಣ ಮೀಸಲಾತಿ ಕೋರುವ ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ ಹಾಗೂ ಹಿಂದುಳಿದ ವರ್ಗಗಳಿಗೆ ಸೇರಿದ ಅಭ್ಯರ್ಥಿಗಳ ಮೀಸಲಾತಿ ಪ್ರಮಾಣ ಪತ್ರಗಳು ತಿರಸ್ಕೃತಗೊಂಡಲ್ಲಿ ಅವರು ಗ್ರಾಮೀಣ ಮೀಸಲಾತಿಗೂ ಅನರ್ಹರಾಗುತ್ತಾರೆ.
7. ಗ್ರಾಮೀಣ ಮೀಸಲಾತಿಯನ್ನು ಕೋರುವ ಸಾಮಾನ್ಯ ವರ್ಗದ ಅಭ್ಯರ್ಥಿಗಳು ಪ್ರಮಾಣಪತ್ರ ನಮೂನೆ–2 ರ ಜೊತೆ ನಮೂನೆ–1 ರಲ್ಲೂ ದೃಢೀಕರಣ ಪತ್ರವನ್ನು ಸಲ್ಲಿಸುವುದು.
8. ಕನ್ನಡ ಮಾಧ್ಯಮ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ನಿಗದಿತ ನಮೂನೆಯಲ್ಲಿ ಕನ್ನಡ ಮಾಧ್ಯಮದಲ್ಲಿ ವ್ಯಾಸಂಗ ಮಾಡಿರುವ ಬಗ್ಗೆ ಸಂಬಂಧಪಟ್ಟ ಶಾಲೆಯ ಮುಖ್ಯೋಪಾಧ್ಯಾಯರ ಸಹಿ ಮತ್ತು ಮೊಹರಿನೊಂದಿಗೆ ಕನ್ನಡ ಮಾಧ್ಯಮ ವ್ಯಾಸಂಗ ಪ್ರಮಾಣಪತ್ರವನ್ನು ಪಡೆದು ಸಲ್ಲಿಸುವುದು.
9. ಅಂಗವಿಕಲ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ವೈದ್ಯಕೀಯ ಪ್ರಮಾಣಪತ್ರವನ್ನು ದಿ:19.11.2005ರ ಅಧಿಕೃತ ಜ್ಞಾಪನಾ ಸಂಖ್ಯೆ:ಸಿಆಸುಇ/115/ಸೇನನಿ/2005 ರಲ್ಲಿ ನಿಗದಿಪಡಿಸಿದ ನಮೂನೆಯಲ್ಲಿ ಸಂಬಂಧಿಸಿದ ತಹಸೀಲ್ದಾರರಿಂದ ಪ್ರಮಾಣಪತ್ರವನ್ನು ಪಡೆದು ಸಲ್ಲಿಸತಕ್ಕದ್ದು.
10. ವಾಹನ ಚಾಲನೆಯ ರಹದಾರಿ (ಆದೇಶ ಜಾರಿಕಾರರ ಹುದ್ದೆಗೆ ಅರ್ಜಿ ಸಲ್ಲಿಸುವ ಅಭ್ಯರ್ಥಿಗಳು ಮಾತ್ರ).
11. ವಿಧವೆಯರು, ಜೀತ ಕಾರ್ಮಿಕರು ಹಾಗೂ ವಯೋಮಿತಿ ರಿಯಾಯಿತಿಗೆ ಅರ್ಹರಾದ ಇನ್ನಿತರರು ವಯೋಮಿತಿ ರಿಯಾಯಿತಿ ಕೋರಲು ಸಕ್ಷಮ ಪ್ರಾಧಿಕಾರದಿಂದ ಪಡೆದ ಪ್ರಮಾಣಪತ್ರವನ್ನು ಸಲ್ಲಿಸುವುದು.

**ಪ್ರಮುಖವಾದ ಸೂಚನೆಗಳು:**

ಈ ಕೆಳಗಿನ ಸಂದರ್ಭಗಳಲ್ಲಿ ನೇಮಕಾತಿಯ ಗರಿಷ್ಠ ವಯೋಮಿತಿಯನ್ನು ಆಯಾ ಅಭ್ಯರ್ಥಿಗಳಿಗೆ ನಮೂದಿಸಿರುವ ಮಟ್ಟಿಗೆ ಹೆಚ್ಚಿಸಲಾಗುವುದು. ಅರ್ಹತಾ ಪರೀಕ್ಷೆಗೆ ಹಾಜರಾಗುವ ಅಭ್ಯರ್ಥಿಗಳು ತಮ್ಮ ಸ್ವಂತ ಖರ್ಚಿನಲ್ಲಿ ಹಾಜರಾಗುವುದು.

1. ಅಭ್ಯರ್ಥಿಯು ಕರ್ನಾಟಕ ರಾಜ್ಯ ಸರ್ಕಾರದಲ್ಲಿ ಅಥವಾ ಸ್ಥಳೀಯ ಪ್ರಾಧಿಕಾರದಲ್ಲಿ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಯಾದ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಗೊಂಡು ಕರ್ನಾಟಕ ರಾಜ್ಯ ಸರ್ಕಾರದ ಸ್ವಾಮ್ಯ ಅಥವಾ ನಿಯಂತ್ರಣದಲ್ಲಿರುವ ನಿಗಮದಲ್ಲಿ ಹುದ್ದೆ ಹೊಂದಿರುವ ಅಥವಾ ಹಿಂದೆ ಹೊಂದಿದ್ದಲ್ಲಿ ಗರಿಷ್ಠ ವಯೋಮಿತಿಯನ್ನು ಅವರು ಎಷ್ಟು ವರ್ಷಗಳ ಅವಧಿಗೆ ಹುದ್ದೆಯಲ್ಲಿ ಸೇವೆ ಸಲ್ಲಿಸಿರುವರೋ ಅಥವಾ ಹಿಂದೆ ಸಲ್ಲಿಸಿದ್ದರೋ ಅಷ್ಟು ವರ್ಷಗಳು ಅಥವಾ 10 ವರ್ಷಗಳ ಅವಧಿ, ಎರಡರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳ ಸಡಿಲಿಕೆಯನ್ನು ನೀಡಲಾಗುವುದು.
2. ಅಭ್ಯರ್ಥಿಯು ಮಾಜಿ ಸೈನಿಕನಾಗಿದ್ದಲ್ಲಿ, ಅವನು ಸಶಸ್ತ್ರ ದಳಗಳಲ್ಲಿ ಎಷ್ಟು ವರ್ಷ ಸೇವೆ ಸಲ್ಲಿಸಿರುವನೋ ಆ ವರ್ಷಗಳಿಗೆ 03 ವರ್ಷಗಳನ್ನು ಸೇರಿಸಿದರೆ ಎಷ್ಟು ವರ್ಷಗಳಾಗುವುವೋ ಅಷ್ಟು ವರ್ಷಗಳು.
3. ಅಭ್ಯರ್ಥಿಯು ಅಂಗವಿಕಲನಾಗಿದ್ದಲ್ಲಿ, ವಿಧವೆಯಾಗಿದ್ದಲ್ಲಿ ಮತ್ತು ಜೀತ ಕಾರ್ಮಿಕನಾಗಿದ್ದಲ್ಲಿ 10 ವರ್ಷಗಳು.
4. ಅಭ್ಯರ್ಥಿಯು ಕರ್ನಾಟಕ ರಾಜ್ಯದಲ್ಲಿರುವ ಭಾರತ ಸರ್ಕಾರದ ಜನಗಣತಿ ಸಂಸ್ಥೆಯಲ್ಲಿ ಈಗ ಹುದ್ದೆಯನ್ನು ಹೊಂದಿದ್ದ ಪಕ್ಷದಲ್ಲಿ ಗರಿಷ್ಠ ವಯೋಮಿತಿಯನ್ನು ಅಭ್ಯರ್ಥಿಯು ಎಷ್ಟು ವರ್ಷಗಳ ಅವಧಿಗೆ ಆ ಹುದ್ದೆಯಲ್ಲಿ ಸೇವೆ ಸಲ್ಲಿಸುತ್ತಿರುವರೋ ಅಥವಾ ಹಿಂದೆ ಸೇವೆ ಸಲ್ಲಿಸಿದ್ದಾರೋ ಅಷ್ಟು ವರ್ಷಗಳ ಅಥವಾ 05 ವರ್ಷಗಳ ಅವಧಿ, ಅದರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳು.
5. ಸೇವೆಯಲ್ಲಿರುವ ಅಭ್ಯರ್ಥಿಗಳು ಅರ್ಜಿಯೊಂದಿಗೆ ತಮ್ಮ ಮೇಲಾಧಿಕಾರಿಗಳಿಂದ ಪಡೆದ ನಿರಾಕ್ಷೇಪಣಾ ಪ್ರಮಾಣ ಪತ್ರವನ್ನು ಲಗತ್ತಿಸತಕ್ಕದ್ದು.
6. ಅಭ್ಯರ್ಥಿಯು ನ್ಯಾಷನಲ್ ಕೆಡೆಟ್ ಕಾರ್ಪ್ಸ್‌ನಲ್ಲಿ ಪೂರ್ಣಕಾಲಿಕ ಪರೀಕ್ಷಕರಾಗಿ ಸೇವೆ ಸಲ್ಲಿಸಿ ಬಿಡುಗಡೆಯಾಗಿರುವ ವ್ಯಕ್ತಿಯಾಗಿದ್ದರೆ ಅಂತಹ ಕೆಡೆಟ್ ಪರೀಕ್ಷಕನಾಗಿ ಸೇವೆ ಸಲ್ಲಿಸಿದ್ದಷ್ಟು ವರ್ಷಗಳು.
7. ಅಭ್ಯರ್ಥಿಯು ರಾಜ್ಯ ಸರ್ಕಾರದಿಂದ ಪುರಸ್ಕೃತವಾದ ಗ್ರಾಮೀಣ ಔದ್ಯಮೀಕರಣ ಯೋಜನೆಯ ಮೇರೆಗೆ ನೇಮಕಗೊಂಡು ಗ್ರಾಮಸಮೂಹ ಪರಿಶೀಲಕರಾಗಿ ಈಗ ಕೆಲಸ ಮಾಡುತ್ತಿದ್ದರೆ ಅಥವಾ ಹಿಂದೆ ಇದ್ದ ಪಕ್ಷದಲ್ಲಿ ಅಂತಹ ಗ್ರಾಮ ಸಮೂಹ ಪರಿಶೀಲಕರಾಗಿ ಸೇವೆ ಸಲ್ಲಿಸಿದ್ದಷ್ಟು ವರ್ಷಗಳು.

**ಇತರೆ ಸೂಚನೆಗಳು:**

1. ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕವು ಸಾರ್ವತ್ರಿಕ ರಜಾ ದಿನವಾಗಿ ಘೋಷಿಸಲ್ಪಟ್ಟರೆ ಆ ದಿನಾಂಕದ ಮಾರನೆಯ ಕೆಲಸದ ದಿನವು ಅರ್ಜಿಗಳನ್ನು ಸ್ವೀಕರಿಸಲು ಕೊನೆಯ ದಿನಾಂಕವಾಗುವುದು.
2. ಒಂದಕ್ಕಿಂತ ಹೆಚ್ಚು ಹುದ್ದೆಗೆ ಅರ್ಜಿ ಸಲ್ಲಿಸುವವರು ಪ್ರತಿ ಹುದ್ದೆಗಳಿಗೂ ಪ್ರತ್ಯೇಕವಾಗಿ ಅರ್ಜಿಗಳನ್ನು ಸಲ್ಲಿಸತಕ್ಕದ್ದು.
3. ಅರ್ಜಿಯಲ್ಲಿ ಮತ್ತು ಲಕೋಟೆಯ ಮೇಲೆ ಹುದ್ದೆಯ ಹೆಸರನ್ನು ಕಡ್ಡಾಯವಾಗಿ ನಮೂದಿಸತಕ್ಕದ್ದು.

4. ಅರ್ಜಿಯೊಂದಿಗೆ 5 ರೂಪಾಯಿ ಅಂಚೆ ಚೀಟಿ (Postal Stamp) ವನ್ನು ಹೊಂದಿರುವ ಸ್ವ-ವಿಳಾಸದ ಲಕೋಟೆಯನ್ನು ಸಲ್ಲಿಸತಕ್ಕದ್ದು.
5. ಅರ್ಜಿಯೊಂದಿಗೆ ಅಭ್ಯರ್ಥಿಗಳು ತಮ್ಮ ಇತ್ತೀಚಿನ ಒಂದು ಭಾವಚಿತ್ರವನ್ನು ಸ್ವದೃಢೀಕರಿಸಿ ಲಗತ್ತಿಸಬೇಕು.
6. ಸಂದರ್ಶನ ಪತ್ರ ಬರದಿರುವ ಅಭ್ಯರ್ಥಿಗಳು ಸಂದರ್ಶನಕ್ಕೆ ಅರ್ಹರಲ್ಲವೆಂದು ಭಾವಿಸಿಕೊಳ್ಳತಕ್ಕದ್ದು.
7. ಆಯ್ಕೆಯ ಸಂಬಂಧವಾಗಿ ಸಂದರ್ಶನಕ್ಕೆ ಅನರ್ಹರಾದ ಅಭ್ಯರ್ಥಿಗಳು ಈ ಕಛೇರಿಯೊಂದಿಗೆ ಯಾವುದೇ ಪತ್ರ ವ್ಯವಹಾರವನ್ನು ನಡೆಸಲು ಆಸ್ಪದವಿರುವುದಿಲ್ಲ.

**ಬಿ.ಎ. ಪಾಟೀಲ್**
**ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು,**
**ಚಿಕ್ಕಮಗಳೂರು.**

**ಅರ್ಜಿ ನಮೂನೆ**

| ಸ್ವದೃಢೀಕರಿಸಿದ ಪಾಸ್‌ಪೋರ್ಟ್ ಅಳತೆಯ ಭಾವಚಿತ್ರವನ್ನು ಅಂಟಿಸಬೇಕು. |
|---|

ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು,
ಚಿಕ್ಕಮಗಳೂರು ಜಿಲ್ಲೆ,
ಚಿಕ್ಕಮಗಳೂರು – ಇವರಿಗೆ:

ಮಾನ್ಯರೇ,

ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರ ಅಧಿಸೂಚನೆ ಸಂಖ್ಯೆಃ **01/2013** ದಿನಾಂಕ: **12–06–2013**ರ ಪ್ರಕಾರ ನಾನು ಕೆಳಕಂಡ ಮಾಹಿತಿಗಳೊಂದಿಗೆ ಶೀಘ್ರಲಿಪಿಗಾರರು/ಬೆರಳಚ್ಚುಗಾರರು/ಬೆರಳಚ್ಚು–ನಕಲುಗಾರರು/ಆದೇಶಜಾರಿಕಾರರು/ಸೇವಕರ ಹುದ್ದೆಗೆ ಈ ಮೂಲಕ ನನ್ನ ವಿವರಗಳೊಂದಿಗೆ ಅರ್ಜಿ ಸಲ್ಲಿಸುತ್ತಿದ್ದೇನೆ.

| | | | | |
|---|---|---|---|---|
| 01 | ಅಭ್ಯರ್ಥಿಯ ಹೆಸರು (ದಪ್ಪ ಅಕ್ಷರಗಳಲ್ಲಿ) | | | |
| 02 | ತಂದೆ / ಗಂಡನ ಹೆಸರು | | | |
| 03 | ತಾಯಿಯ ಹೆಸರು | | | |
| 04 | ಜನ್ಮ ದಿನಾಂಕ | | | |
| 05 | ವಯಸ್ಸು (ಅರ್ಜಿಯನ್ನು ಸ್ವೀಕರಿಸಲು ನಿಗದಿಪಡಿಸಿರುವ ಕೊನೆಯ ದಿನಾಂಕದಂದು ಅಭ್ಯರ್ಥಿಯ ವಯಸ್ಸು) | ವರ್ಷಗಳು | ತಿಂಗಳುಗಳು | ದಿನಗಳು |
| | | | | |
| 06 | ಅಭ್ಯರ್ಥಿಯ ಖಾಯಂ ವಿಳಾಸ ಮತ್ತು ದೂರವಾಣಿ ಸಂಖ್ಯೆ | | | |
| 07 | ಲಿಂಗ | ಪುರುಷ / ಮಹಿಳೆ | | |
| 08 | ರಾಷ್ಟ್ರೀಯತೆ ಮತ್ತು ಧರ್ಮ | | | |
| 09 | ಜಾತಿ / ಉಪಜಾತಿ | | | |
| 10 | ವಿವಾಹಿತರಾದಲ್ಲಿ ಒಬ್ಬರಿಗಿಂತ ಹೆಚ್ಚು ಜೀವಂತ ಗಂಡ ಅಥವಾ ಹೆಂಡತಿ ಇದ್ದಾರೆಯೇ? | | | |
| 11 | ನೀವು ಯಾವುದಾದರೂ ಕ್ರಿಮಿನಲ್ ಮೊಕದ್ದಮೆಯಲ್ಲಿ ಭಾಗಿಯಾಗಿದ್ದೀರ? | | | |
| 12 | ನೀವು ಸರ್ಕಾರಿ ಸೇವೆಯಿಂದ ಅಥವಾ ಇನ್ನಾವುದಾದರೂ ಸೇವೆಯಿಂದ ವಜಾ ಆಗಿದ್ದೀರ ಅಥವಾ ತೆಗೆದುಹಾಕಲ್ಪಟ್ಟಿದ್ದೀರ? | | | |
| 13 | ನೀವು ಪ್ರಸ್ತುತ ಸರ್ಕಾರಿ ಸೇವೆಯಲ್ಲಿರುವಿರಾ? (ಸರ್ಕಾರಿ ಸೇವೆಯಲ್ಲಿದ್ದಲ್ಲಿ, ನೇಮಕಾತಿ ಪ್ರಾಧಿಕಾರದಿಂದ ಪಡೆದ ನಿರಾಕ್ಷೇಪಣಾ ಪತ್ರದ ಪ್ರತಿಯನ್ನು ಕಡ್ಡಾಯವಾಗಿ ಲಗತ್ತಿಸಬೇಕು) | ಹೌದು ( ) | ಇಲ್ಲ ( ) | |

<table>
<tr><td rowspan="4">14</td><td rowspan="4">ಕೋರುವ ಮೀಸಲಾತಿಗಳು<br>(ಕೋರುವ ಮೀಸಲಾತಿಯನ್ನು ✓ಚಿಹ್ನೆ ಹಾಕುವುದರ ಮೂಲಕ ಗುರುತಿಸಿ ಪ್ರಮಾಣಪತ್ರದ ಸ್ವಯಂ ದೃಢೀಕೃತ ನಕಲನ್ನು ಲಗತ್ತಿಸಬೇಕು)</td><td>ಸಾಮಾನ್ಯ</td><td>ಪ.ಜಾತಿ</td><td>ಪ.ಪಂಗಡ</td><td>ಪ್ರವರ್ಗ–1</td></tr>
<tr><td></td><td></td><td></td><td></td></tr>
<tr><td>2–ಎ</td><td>2–ಬಿ</td><td>3–ಎ</td><td>3–ಬಿ</td></tr>
<tr><td></td><td></td><td></td><td></td></tr>
</table>

<table>
<tr><td rowspan="2">15</td><td rowspan="2">ನೀವು ಈ ಯಾವುದಾದರೂ ಮೀಸಲಾತಿ ಅಡಿಯಲ್ಲಿ ಬರುತ್ತೀರ?<br>(ಸೇರುವ ಮೀಸಲಾತಿಯನ್ನು ✓ಚಿಹ್ನೆ ಹಾಕುವುದರ ಮೂಲಕ ಗುರುತಿಸಿ ಪ್ರಮಾಣಪತ್ರದ ಸ್ವಯಂ ದೃಢೀಕೃತ ನಕಲನ್ನು ಲಗತ್ತಿಸಬೇಕು)</td><td>ಗ್ರಾಮೀಣ</td><td>ಕ.ಮಾ.ಅ.</td><td>ಮಾ.ಸೈ.</td><td>ಅಂ.ಅ.</td><td>ಯೋ.ನಿ.ಅ.</td></tr>
<tr><td></td><td></td><td></td><td></td><td></td></tr>
</table>

<table>
<tr><td rowspan="8">16</td><td>ಶೈಕ್ಷಣಿಕ ವಿದ್ಯಾರ್ಹತೆ<br>(ಅನ್ವಯಿಸುವ ವಿದ್ಯಾರ್ಹತೆಯ ಅಂಕಣಗಳನ್ನು ಮಾತ್ರ ಭರ್ತಿ ಮಾಡುವುದು)<br>(ಸ್ವಯಂ ದೃಢೀಕೃತ ಪ್ರಮಾಣ ಪತ್ರಗಳನ್ನು ಸಲ್ಲಿಸತಕ್ಕದ್ದು)</td><td>ಉತ್ತೀರ್ಣ ಹೊಂದಿದ ವರ್ಷ</td><td>ಗರಿಷ್ಠ ಅಂಕಗಳು</td><td>ಗಳಿಸಿದ ಅಂಕಗಳು</td><td>ಶೇಕಡಾವಾರು ಅಂಕಗಳು</td></tr>
<tr><td>ಎಸ್‌ಎಸ್‌ಎಲ್‌ಸಿ</td><td></td><td></td><td></td><td></td></tr>
<tr><td>ಕನ್ನಡ ಬೆರಳಚ್ಚು (ಕಿರಿಯ ಶ್ರೇಣಿ)</td><td></td><td></td><td></td><td></td></tr>
<tr><td>ಆಂಗ್ಲ ಬೆರಳಚ್ಚು (ಕಿರಿಯ ಶ್ರೇಣಿ)</td><td></td><td></td><td></td><td></td></tr>
<tr><td>ಕನ್ನಡ ಬೆರಳಚ್ಚು (ಹಿರಿಯ ಶ್ರೇಣಿ)</td><td></td><td></td><td></td><td></td></tr>
<tr><td>ಆಂಗ್ಲ ಬೆರಳಚ್ಚು (ಹಿರಿಯ ಶ್ರೇಣಿ)</td><td></td><td></td><td></td><td></td></tr>
<tr><td>ಕನ್ನಡ ಶೀಘ್ರಲಿಪಿ (ಹಿರಿಯ ಶ್ರೇಣಿ)</td><td></td><td></td><td></td><td></td></tr>
<tr><td>ಆಂಗ್ಲ ಶೀಘ್ರಲಿಪಿ (ಹಿರಿಯ ಶ್ರೇಣಿ)</td><td></td><td></td><td></td><td></td></tr>
</table>

**ಸೂಚನೆ:** ಅಭ್ಯರ್ಥಿಗಳು ಎಲ್ಲಾ ಕಾಲಂಗಳನ್ನು ಖಡ್ಡಾಯವಾಗಿ ಭರ್ತಿ ಮಾಡತಕ್ಕದ್ದು.

**ಘೋಷಣೆ**

ಈ ಮೇಲೆ ನಮೂದಿಸಿರುವ ಮಾಹಿತಿ ಮತ್ತು ವಿವರಗಳು ಸತ್ಯವಾಗಿದ್ದು ಒಂದು ವೇಳೆ ಅವು ಅಸತ್ಯವೆಂದು ಕಂಡು ಬಂದಲ್ಲಿ ತಾವು ತೆಗೆದುಕೊಳ್ಳುವ ತೀರ್ಮಾನಗಳಿಗೆ ಬದ್ಧನಾಗಿರುತ್ತೇನೆ / ಬದ್ಧಳಾಗಿರುತ್ತೇನೆ. ನಾನು ಆಯ್ಕೆಗೊಂಡ ಪಕ್ಷದಲ್ಲಿ ಚಿಕ್ಕಮಗಳೂರು ಜಿಲ್ಲೆಯ ಯಾವುದೇ ನ್ಯಾಯಾಲಯಗಳಲ್ಲಿ ಕರ್ತವ್ಯ ನಿರ್ವಹಿಸಲು ಸಿದ್ಧನಿರುತ್ತೇನೆ/ಸಿದ್ಧಳಿರುತ್ತೇನೆ.

ಸ್ಥಳ:

ದಿನಾಂಕ:

**P.R. 81** **ಅಭ್ಯರ್ಥಿಯ ಸಹಿ**

## FORM-I

(See Rule 9)

**OFFICE OF THE SUPERINTENDENT OF POLICE, BIJAPUR**

**NOTIFICATION**

**Dated : 24-06-2013**

**Shri/Smt. Gurappa Manu Lamani** working as CPC-1173 in the Police Department of /Office of The Superintendent of Police, Bijapur District is permitted to change his/her name to **Gurappa Manu Nayak.**

**P.D. C/N 72** Superintendent of Police
**SC - 5** Bijapur

## FORM-I

(See Rule 9)

**OFFICE OF THE SUPERINTENDENT OF POLICE, BIJAPUR**

**NOTIFICATION**

**Dated : 24-06-2013**

**Shri/Smt. Sharanappa Lalappa Madar** working as CPC-1203 in the Police Department of /Office of The Superintendent of Police, Bijapur District is permitted to change his/her name to **Sharanappa Lalappa Aiholli.**

**P.D. C/n 75** Superintendent of Police
**SC - 5** Bijapur

## FORM-I

(See Rule 9)

**OFFICE OF THE DEPUTY DIRECTOR, BAGALKOT**

**NOTIFICATION**

**Dated : 5-06-2013**

**Shri/Smt. Roopalappa Joolappa Lamani** working as Assistant Teacher in the Education Department of /Office of The Government Higher Primary School, Budni P.D. Mahalingapur Taluk Mudhol, District Bagalkot, is permitted to change his/her name to **Roopasingh Jeevappa Datta.**

**P.D. C/N 73**
**SC - 5**

ಉಪ ನಿರ್ದೇಶಕರು (ಆಡಳಿತ)
ಸಾರ್ವಜನಿಕ ಶಿಕ್ಷಣ ಇಲಾಖೆ, ಬಾಗಲಕೋಟ

## FORM-IV

(See Rule 12)

**NOTICE**

It is hereby notified that the undersigned has changed his/her name from **MANJUNATH KAMALPUR** to **MANJUNATH THIPPANNA HAVERI.**

**P.D. C/N 74**
**SC - 5**

**MANJUNATH KAMLAPUR**

## FORM-I

(See Rule 9)

**OFFICE OF THE COP HUBLI-DHARWAD**

**NOTIFICATION**

**Dated : 26-06-2013**

**Shri/Smt. Sapna Madiwalappa Chalawadi** working as Women Police Constable in the Police Department of /Office of The Ashok Nagar Police Station, Hubli is permitted to change his/her name to **Namita Venkatesh Doddamani.**

**P.D. C/N 76**
**SC - 5**

Police Commissioner
Hubli-Dharwad

## FORM-I

(See Rule 9)

**OFFICE OF THE DEPUTY DIRECTOR, BAGALKOT**

**NOTIFICATION**

**Dated : 5-06-2013**

**Shri/Smt. Shankreppa Shivappa Harijan** working as Assistant Teacher in the Education Department of Office of The Government Lower Primary School, D.P.E.P. Labour Colony Sameerwadi Taluk Mudhol, District Bagalkot, is permitted to change his/her name to **Shankar Shivappa Hadimani.**

**P.D. C/n 77**
**SC - 5**

ಉಪ ನಿರ್ದೇಶಕರು (ಆಡಳಿತ)
ಸಾರ್ವಜನಿಕ ಶಿಕ್ಷಣ ಇಲಾಖೆ, ಬಾಗಲಕೋಟ

## ನಮೂನೆ–1

**(ನಿಯಮ–9)**

**ಕಾರ್ಯಾಲಯ ಉಪ–ಕಾರಾಗೃಹ ಹುಬ್ಬಳ್ಳಿ**

**ಅಧಿಸೂಚನೆ**

**ಶ್ರೀ/ಶ್ರೀಮತಿ ಸಾವಿತ್ರಿ ಕತ್ತಿ** ಇವರು ಕಾರಾಗೃಹ ಇಲಾಖೆಯ ಕಾರ್ಯಾಲಯದ ಕಛೇರಿಯಲ್ಲಿ ದ್ವಿತೀಯ ದರ್ಜೆ ಸಹಾಯಕರು ಉಪಕಾರಾಗೃಹ ಹುಬ್ಬಳ್ಳಿಯ, ಇಲ್ಲಿ ಕಾರ್ಯ ನಿರ್ವಹಿಸುತ್ತಿದ್ದು, ಇವರ ಹೆಸರು ಬದಲಾವಣೆ ಮಾಡಲು ಕೋರಿರುತ್ತಾರೆ. ಅದರಂತೆ ಸದರಿ ನೌಕರರ ಹೆಸರನ್ನು **ಶ್ರೀ/ಶ್ರೀಮತಿ ಸಾವಿತ್ರಿ ಕೊಂ. ಬಸವರಾಜ ದಿಂಡವಾರ** ಎಂದು ಬದಲಾವಣೆಗೆ ಅನುಮತಿ ನೀಡಲಾಗಿದೆ.

**P.D. C/n 78**
**SC - 5**

ಕರ್ನಾಟಕದ ಕಾರಾಗೃಹಗಳ ಉಪ ಮಹಾ ನಿರೀಕ್ಷಕರು
ಬೆಂಗಳೂರು

**ಅಧ್ಯಕ್ಷರು, ಗ್ರಾಮಲೆಕ್ಕಿಗರ ನೇಮಕಾತಿ ಮತ್ತು ಆಯ್ಕೆ ಪ್ರಾಧಿಕಾರ ಹಾಗೂ ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ, ಚಿಕ್ಕಬಳ್ಳಾಪುರ ರವರ ಕಾರ್ಯಾಲಯ,**

**ಸಂಖ್ಯೆ: ಸಿಬ್ಬಂದಿ(1)ಸಿಆರ್.19/2013–14 ದಿನಾಂಕ: 23/06/2013**

**ಅಧಿಸೂಚನೆ**

**ವಿಷಯ :** ಚಿಕ್ಕಬಳ್ಳಾಪುರ ಜಿಲ್ಲಾ ಕಂದಾಯ ಘಟಕದಲ್ಲಿ ವಿವಿಧ ಕಾರಣಗಳಿಂದ ತೆರವಾಗಿರುವ ಹಾಗೂ ತೆರವಾಗುವ ಗ್ರಾಮಲೆಕ್ಕಾಧಿಕಾರಿಗಳ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ತುಂಬುವ ಬಗ್ಗೆ.

ಚಿಕ್ಕಬಳ್ಳಾಪುರ ಜಿಲ್ಲೆಯ ಕಂದಾಯ ಘಟಕದಲ್ಲಿ ವಿವಿಧ ಕಾರಣಗಳಿಂದ ಖಾಲಿ ಇರುವ ಹಾಗು ತೆರವಾಗಲಿರುವ 80 ಗ್ರಾಮಲೆಕ್ಕಾಧಿಕಾರಿಗಳ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ತುಂಬಲು ಅರ್ಜಿಗಳನ್ನು ಅಹ್ವಾನಿಸಲಾಗಿದೆ. ಆಸಕ್ತ ಅರ್ಹ ಅಭ್ಯರ್ಥಿಗಳು ಅರ್ಜಿಗಳನ್ನು ಆನ್‌ಲೈನ್‌ನಲ್ಲಿ ಭರ್ತಿ ಮಾಡಿ, ದಿನಾಂಕ: 26/07/2013 ರ ಸಂಜೆ 5–30 ಗಂಟೆಯ ಒಳಗಾಗಿ ಸಲ್ಲಿಸಬಹುದಾಗಿರುತ್ತದೆ. ಹುದ್ದೆಗಳ ಸಂಖ್ಯೆ ವೇತನಶ್ರೇಣಿ, ಅರ್ಜಿ ಶುಲ್ಕ, ಮೀಸಲಾತಿ ವಿವರಗಳು ಇತ್ಯಾಧಿ ಎಲ್ಲಾ ಷರತ್ತುಗಳನ್ನು ಪ್ರತ್ಯೇಕವಾಗಿ ಅನುಬಂಧದಲ್ಲಿ ವಿವರಿಸಲಾಗಿದೆ. ಈ ಮಾಹಿತಿಯನ್ನು http://cbpur-va.kar.nic.in ವೆಬ್‌ಸೈಟ್ ನಲ್ಲಿಯೂ ಸಹ ಅಪ್‌ಲೋಡ್ ಮಾಡಲಾಗಿರುತ್ತದೆ.

**ಅಧ್ಯಕ್ಷರು**
ಗ್ರಾಮಲೆಕ್ಕಿಗರ ನೇಮಕಾತಿ ಮತ್ತು ಆಯ್ಕೆ ಪ್ರಾಧಿಕಾರ
ಹಾಗೂ ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ.

**ಅಧಿಸೂಚನೆ ಸಂಖ್ಯೆ: ಸಿಬ್ಬಂದಿ(1)ಸಿಆರ್.19/2013–14 ಕ್ಕೆ ಅನುಬಂಧ**

ಚಿಕ್ಕಬಳ್ಳಾಪುರ ಜಿಲ್ಲೆ, ಕಂದಾಯ ಘಟಕದಲ್ಲಿ ಖಾಲಿ ಇರುವ ಗ್ರಾಮಲೆಕ್ಕಾಧಿಕಾರಿಗಳ ಹುದ್ದೆಗಳನ್ನು ವರ್ಗೀಕರಣ ಮತ್ತು ಮೀಸಲಾತಿ ಅನ್ವಯ ಕರ್ನಾಟಕ ನಾಗರೀಕ ಸೇವೆಗಳು (Revenue Sub-ordinate Branch) (Cadre and Recruitment) (Amendment) ನಿಯಮಗಳು–2008 ರ ನಿಯಮ–2 ರನ್ವಯ ಮತ್ತು 2009 ರನ್ವಯ ನೇರ ನೇಮಕಾತಿ ಮೂಲಕ ಭರ್ತಿ ಮಾಡಲು ಅರ್ಹ ಹಾಗೂ ಆಸಕ್ತ ಅಭ್ಯರ್ಥಿಗಳಿಂದ ಅರ್ಜಿಗಳನ್ನು ಆನ್‌ಲೈನ್‌ನಲ್ಲಿ ಆಹ್ವಾನಿಸಲಾಗಿದೆ.

**1. ಹುದ್ದೆಗಳ ಸಂಖ್ಯಾ ವಿವರ ಮತ್ತು ವಿಧ್ಯಾರ್ಹತೆ :**

| ಹುದ್ದೆಯ ಹೆಸರು | ಒಟ್ಟು ಹುದ್ದೆ | ವಿದ್ಯಾರ್ಹತೆ |
|---|---|---|
| ಗ್ರಾಮಲೆಕ್ಕಾಧಿಕಾರಿ | 80 | ಪಿ.ಯು.ಸಿ. ಅಥವಾ (ಸಿಬಿಎಸ್‌ಇ/ ಐಸಿಎಸ್‌ಇ) 12ನೇ ತರಗತಿ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು ಹಾಗೂ ಕನ್ನಡ ಮತ್ತು ಆಂಗ್ಲ ಭಾಷೆಯ ಗಣಕಯಂತ್ರ ನಿರ್ವಹಣೆ (MS Office) ಬಗ್ಗೆ ಪ್ರಮಾಣ ಪತ್ರಗಳನ್ನು ಅರ್ಜಿ ಸಲ್ಲಿಸುವ ದಿನಾಂಕಕ್ಕೆ ಮುಂಚಿತವಾಗಿ ಹೊಂದಿರಬೇಕು. ಮುಕ್ತ ವಿದ್ಯಾಲಯದಿಂದ ನೀಡಲಾದ ಪ್ರಮಾಣ ಪತ್ರ ಪರಿಗಣಿಸಲಾಗುವುದಿಲ್ಲ. |

**2. ವೇತನ ಶ್ರೇಣಿ : ರೂ. 11600–200–12000–250–13000–300–14200–350–15600–400–17200–450–19000–500–21000**

**3. ಮೀಸಲಾತಿ ವರ್ಗೀಕರಣ :**

**ಒಟ್ಟು 80 ಹುದ್ದೆಗಳು 75ನೇ ರೋಷ್ಟರ್ ಬಿಂದುವಿನಿಂದ 153 ರವರೆಗೆ**

| ಕ್ರ. ಸಂ. | ಮೀಸಲಾತಿ | ಸಾಮಾನ್ಯ | ಮಹಿಳೆ | ಗ್ರಾಮೀಣ | ಅಂಗವಿಕಲ | ಮಾಜಿಸೈನಿಕ | ಕನ್ನಡ ಮಾಧ್ಯಮ | ಯೋಜನಾ ನಿರಾಶ್ರಿತರು | ಒಟ್ಟು |
|---|---|---|---|---|---|---|---|---|---|
| 1 | ಪರಿಶಿಷ್ಟ ಜಾತಿ | 3 | 4 | 3 | – | 1 | 1 | 1 | 13 |
| 2 | ಪರಿಶಿಷ್ಟ ಪಂಗಡ | – | 1 | – | 1 | – | – | – | 2 |
| 3 | ಪ್ರವರ್ಗ–1 | – | 1 | 1 | 1 | – | – | – | 3 |
| 4 | ಪ್ರವರ್ಗ–2(ಎ) | 2 | 3 | 3 | – | 1 | 1 | 2 | 12 |
| 5 | ಪ್ರವರ್ಗ–2(ಬಿ) | – | 1 | 1 | 1 | – | – | – | 3 |
| 6 | ಪ್ರವರ್ಗ–3(ಎ) | – | 1 | 1 | 1 | – | – | – | 3 |
| 7 | ಪ್ರವರ್ಗ–3(ಬಿ) | 1 | 2 | 1 | – | – | – | – | 4 |
| 8 | ಸಾಮಾನ್ಯ | 8 | 12 | 10 | 2 | 4 | 2 | 2 | 40 |
| | **ಒಟ್ಟು** | **14** | **25** | **20** | **6** | **6** | **4** | **5** | **80** |

4. ಅರ್ಹ ಅಭ್ಯರ್ಥಿಗಳು ಆನ್‌ಲೈನ್ (online) ಮೂಲಕ ಮಾತ್ರವೇ ಅರ್ಜಿಯನ್ನು ಸಲ್ಲಿಸಬೇಕಾಗಿರುತ್ತದೆ. ಅರ್ಜಿಯನ್ನು ಜಿಲ್ಲಾಧಿಕಾರಿಗಳ ಕಛೇರಿಯಿಂದ ಒದಗಿಸಲಾಗುವುದಿಲ್ಲ ಹಾಗೂ ಯಾವುದೇ ಕಾರಣಕ್ಕೂ ಸಹ ನೋಂದಾಯಿತ/ಸಾಮಾನ್ಯ ಅಂಚೆ, ಕೊರಿಯರ್ ಅಥವಾ ಇಮೇಲ್ ಮೂಲಕ ಸಲ್ಲಿಸುವ ಅರ್ಜಿಗಳನ್ನು ಪರಿಗಣಿಸಲಾಗುವುದಿಲ್ಲ. ಅಭ್ಯರ್ಥಿಯು ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ ರವರ ಅಧಿಕೃತ ವೆಬ್ ಸೈಟ್ http://cbpur-va.kar.nic.in ನ ಆನ್‌ಲೈನ್ ಮುಖಾಂತರ ಗ್ರಾಮಲೆಕ್ಕಿಗರ ನೇರನೇಮಕಾತಿ ಅರ್ಜಿ ತುಂಬುವುದು ರ ಮೇಲೆ ಕ್ಲಿಕ್ ಮಾಡಿದಾಗ ತೆರೆದ ಕಂಪ್ಯೂಟರ್ ಪರದೆಯ ಮೇಲೆ ಅರ್ಜಿಯನ್ನು ತುಂಬಬೇಕು. ಅರ್ಜಿಯನ್ನು ಭರ್ತಿ ಮಾಡಿದ ನಂತರ ಅಭ್ಯರ್ಥಿಯು submit button ನ್ನು ಒತ್ತಿದರೆ ಅರ್ಜಿ ಸಂಖ್ಯೆ (reference number) ಉತ್ಪಾದನೆಯಾಗುತ್ತದೆ. ಆನ್‌ಲೈನ್ ಅರ್ಜಿಯನ್ನು ಭರ್ತಿ ಮಾಡಿದ ನಂತರ ಅಭ್ಯರ್ಥಿಗಳು ಸ್ವೀಕೃತಿ ಪತ್ರ (Acknowledgement Slip) ಮತ್ತು ಚಲನ್‌ನ ದ್ವಿಪ್ರತಿಗಳನ್ನು ತೆಗೆದುಕೊಳ್ಳತಕ್ಕದ್ದು. ಈ ಚಲನ್ನನ್ನು ಅರ್ಜಿ ಶುಲ್ಕದೊಂದಿಗೆ ಸ್ಟೇಟ್ ಬ್ಯಾಂಕ್ ಆಫ್ ಮೈಸೂರ್‌ನ ಯಾವುದೇ ಶಾಖೆಯಲ್ಲಿ ಪಾವತಿಸಬಹುದು. ಪಾವತಿಸುವಾಗ ಚಲನ್‌ನಲ್ಲಿ ಅರ್ಜಿಯ ಸಂಖ್ಯೆ (reference number) ಮತ್ತು ಅಭ್ಯರ್ಥಿಯ ಹೆಸರು ಸರಿಯಾಗಿ ನಮೂದಾಗಿದೆಯೇ? ಎಂದು ಅಭ್ಯರ್ಥಿಯು ಪರಿಶೀಲಿಸಿ ದೃಢಪಡಿಸಿಕೊಳ್ಳತಕ್ಕದ್ದು. ಅಭ್ಯರ್ಥಿಗಳು ಸ್ವೀಕೃತಿ ಪತ್ರವನ್ನು ಮತ್ತು ಚಲನ್‌ಪಾವತಿಯ ಒಂದು ಪ್ರತಿಯನ್ನು ಕಡ್ಡಾಯವಾಗಿ ತಮ್ಮ ಬಳಿ ಇರಿಸಿಕೊಳ್ಳತಕ್ಕದ್ದು. ಅರ್ಜಿ ಶುಲ್ಕದ ಜೊತೆಗೆ ಬ್ಯಾಂಕ್ ಸರ್ವೀಸ್ ಚಾರ್ಜ್‌ನ್ನು ಸಹಾ ಅಭ್ಯರ್ಥಿಗಳು ಬ್ಯಾಂಕ್‌ಗೆ ಪಾವತಿಸತಕ್ಕದ್ದು. ಈ ದಾಖಲೆಗಳನ್ನು ಅಭ್ಯರ್ಥಿಗಳ ಮೂಲ ದಾಖಲೆಗಳ ಪರಿಶೀಲನೆಗೆ ನಿಗಧಿಪಡಿಸಿದ ದಿನಾಂಕದಂದು ಹಾಜರುಪಡಿಸತಕ್ಕದ್ದು.

**ಅರ್ಜಿ ಶುಲ್ಕದ ವಿವರ :** ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ, ಪ್ರವರ್ಗ–1 ಹಾಗೂ ಮಹಿಳಾ ಅಭ್ಯರ್ಥಿಗಳಿಗೆ ರೂ. 100/– ಹಾಗೂ ಇತರರಿಗೆ ರೂ. 200/– ಗಳನ್ನು ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ ರವರ State Bank of Mysore, Chickballapur ಶಾಖೆಯಲ್ಲಿನ ಉಳಿತಾಯ ಖಾತೆ ಸಂಖ್ಯೆ :**64030323576 ಗೆ** (IFSC codeSBMY0040082) ಅರ್ಜಿ ಸಲ್ಲಿಸಲು ನಿಗಧಿಪಡಿಸಿದ ಕೊನೆಯ ದಿನಾಂಕಕ್ಕೆ ಮುಂಚೆ ಪಾವತಿ ಮಾಡಿ ಚಲನ್ ಸಂಖ್ಯೆಯನ್ನು ಅರ್ಜಿಯಲ್ಲಿ ದಿನಾಂಕದ ಸಹಿತ ತಪ್ಪದೆ ನಮೂದಿಸುವುದು. ನಿಗಧಿತ ಶುಲ್ಕ ಪಾವತಿಸದ ಅರ್ಜಿಗಳನ್ನು ತಿರಸ್ಕರಿಸಲಾಗುವುದು.

**ಅನ್‌ಲೈನ್ ಮೂಲಕ ಶುಲ್ಕದೊಂದಿಗೆ ಅರ್ಜಿ ಸಲ್ಲಿಸಲು ಕೊನೆಯ ದಿನಾಂಕ: 26/07/2013 ಆಗಿರುತ್ತದೆ.**

5. **ವಯೋಮಿತಿ** : ಅರ್ಜಿಗಳನ್ನು ಸಲ್ಲಿಸಲು ನಿಗಧಿಪಡಿಸಿದ ಕೊನೆಯ ದಿನಾಂಕದಂದು ಅಭ್ಯರ್ಥಿಯು ಕನಿಷ್ಟ 18 ವರ್ಷ ವಯಸ್ಸು ಪೂರೈಸಿರತಕ್ಕದ್ದು. ಗರಿಷ್ಟ ವಯೋಮಿತಿ ಈ ಕೆಳಕಂಡಂತಿರತಕ್ಕದ್ದು.

| | |
|---|---|
| ಸಾಮಾನ್ಯ ವರ್ಗ | 35 ವರ್ಷ |
| 2ಎ, 2ಬಿ, 3ಎ, 3ಬಿ | 38 ವರ್ಷ |
| ಪರಿಶಿಷ್ಟ ಜಾತಿ/ ಪರಿಶಿಷ್ಟ ಪಂಗಡ/ ಪ್ರವರ್ಗ–1 | 40 ವರ್ಷ |
| ವಿಧವೆಯರು/ಅಂಗವಿಕಲ | ಚಾಲ್ತಿಯಲ್ಲಿ ನಿಗಧಿಪಡಿಸಿರುವ ವಯೋಮಿತಿಗೆ 10 ವರ್ಷ ಹೆಚ್ಚಿಗೆ ಸೇರಿಸಿಕೊಳ್ಳಲಾಗುವುದು |
| ಮಾಜಿ ಸೈನಿಕರು | ಸಶಸ್ತ್ರ ದಳದಲ್ಲಿ ಎಷ್ಟು ವರ್ಷ ಸೇವೆ ಸಲ್ಲಿಸಿರುವವರೋ ಅದಕ್ಕೆ 3 ವರ್ಷಗಳನ್ನು ಸೇರಿಸಿದರೆ ಎಷ್ಟು ವರ್ಷಗಳಾಗುವುದೋ ಅಷ್ಟು ವರ್ಷ |

ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ವಿದ್ಯಾರ್ಹತೆಯ ಪ್ರಮಾಣ ಪತ್ರದಲ್ಲಿ ನಮೂದಿಸಿರುವಂತೆ ಜನ್ಮ ದಿನಾಂಕವನ್ನು ಪರಿಗಣಿಸಲಾಗುವುದು. ಇತರೆ ಯಾವುದೇ ದಾಖಲೆಗಳನ್ನು ಪರಿಗಣಿಸಲಾಗುವುದಿಲ್ಲ.

ಕರ್ನಾಟಕ ಸರ್ಕಾರಿ ಸೇವಾ (ಸಾಮಾನ್ಯ ನೇಮಕಾತಿ) 1977 ರ ನಿಯಮಾವಳಿಗಳ ನಿಯಮ 6 ರಂತೆ ಗರಿಷ್ಟ ವಯೋಮಿತಿಯನ್ನು ಈ ಮುಂದಿನ ಪ್ರಕರಣಗಳಲ್ಲಿ ಮುಂದೆ ಹೇಳಿರುವಷ್ಟರ ಮಟ್ಟಿಗೆ ಹೆಚ್ಚಿಸಲು ಅವಕಾಶವಿದೆ.

ಎ) ಸರ್ಕಾರ ಅಥವಾ ಸ್ಥಳೀಯ ಪ್ರಾಧಿಕಾರ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪಿಸಲಾದ ಅಥವಾ ರಾಜ್ಯ ಅಧಿನಿಯಮದ ಅಥವಾ ಕೇಂದ್ರ ಅಧಿನಿಯಮದ ಅಡಿಯಲ್ಲಿ ಸರ್ಕಾರದಿಂದ ಸ್ಥಾಪಿತವಾಗಿದ್ದು ಮತ್ತು ಸರ್ಕಾರವು ಒಡೆತನ ಹೊಂದಿರುವ ಅಥವಾ ನಿಯಂತ್ರಣ ಹೊಂದಿರುವ ನಿಗಮದ ಅಡಿಯಲ್ಲಿ ಹುದ್ದೆಯನ್ನು ಧಾರಣ ಮಾಡಿರುವ ಅಥವಾ ಧಾರಣ ಮಾಡಿದ ಅಭ್ಯರ್ಥಿಯ ಸಂದರ್ಭದಲ್ಲಿ ಆತ ಅಂಥ ಹುದ್ದೆಯನ್ನು ಧಾರಣೆ ಮಾಡಿರುವಷ್ಟು ಅಥವಾ ಧಾರಣೆ ಮಾಡಿದಷ್ಟು ಅಥವಾ (ಹತ್ತು) ವರ್ಷಗಳು ಇವುಗಳಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳು.

ಬಿ) ಅಂಗವಿಕಲನಾಗಿರುವ ಅಭ್ಯರ್ಥಿಯ ಸಂದರ್ಭದಲ್ಲಿ ಹತ್ತು ವರ್ಷಗಳು.

ಸಿ) ಈ ರಾಜ್ಯದಲ್ಲಿರುವ ಭಾರತ ಸರ್ಕಾರ ಜನಗಣತಿ ಸಂಸ್ಥೆಯಲ್ಲಿ ಹುದ್ದೆಯನ್ನು ಧಾರಣೆ ಮಾಡಿರುವ ಅಥವಾ ಧಾರಣ ಮಾಡಿದ್ದ ಅಭ್ಯರ್ಥಿಯ ಸಂದರ್ಭದಲ್ಲಿ ಅಂಥ ಹುದ್ದೆಯನ್ನು ಆತನು ಧಾರಣೆ ಮಾಡಿರುವಷ್ಟು ಅಥವಾ ಧಾರಣೆ ಮಾಡಿದಷ್ಟು ವರ್ಷಗಳು ಅಥವಾ ಐದು ವರ್ಷಗಳು ಇವುಗಳಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳು.

ಡಿ) ಅಭ್ಯರ್ಥಿ ವಿಧವೆಯಾಗಿರುವ ಸಂದರ್ಭದಲ್ಲಿ ಹತ್ತು ವರ್ಷಗಳು.

ಇ) ಜೀತ ಕಾರ್ಮಿಕವಾಗಿದ್ದ ಅಭ್ಯರ್ಥಿಯ ಸಂದರ್ಭದಲ್ಲಿ ಹತ್ತು ವರ್ಷಗಳು.

ಎಫ್) **ಮಾಜಿ ಸೈನಿಕರು :** ಅಭ್ಯರ್ಥಿಯು ಮಾಜಿ ಸೈನಿಕನಾಗಿದ್ದಲ್ಲಿ ಅವರು ಸಶಸ್ತ್ರ ದಳದಲ್ಲಿ ಎಷ್ಟು ವರ್ಷ ಸೇವೆ ಸಲ್ಲಿಸಿರುವರೊ ಅಷ್ಟು ವರ್ಷಗಳಿಗೆ ಮೂರು ವರ್ಷಗಳನ್ನು ಸೇರಿಸಿದರೆ ಎಷ್ಟು ವರ್ಷಗಳಾಗುವುದೋ ಅಷ್ಟು ವರ್ಷಗಳು.

ಅ) ಮಾಜಿ ಸೈನಿಕ ಎಂದರೆ ಸಶಸ್ತ್ರ ದಳಗಳಾದ ನಿಯಮಿತ ಭೂದಳ, ನೌಕಾದಳ ಮತ್ತು ವಾಯುದಳದಲ್ಲಿ ಯಾವುದೇ ಶ್ರೇಣಿಯಲ್ಲಿ (ಯೋಧ ಅಥವಾ ಯೋಧನಾಗಿಲ್ಲದೆ) ಸೇವೆ ಸಲ್ಲಿಸಿದ ವ್ಯಕ್ತಿ ಎಂದು ಅರ್ಥ. ಅಂದರೆ ಡಿಫೆನ್ಸ್, ಸೆಕ್ಯೂರಿಟಿಕೋರ್, ಜನರಲ್ ರಿಸರ್ವ್ ಇಂಜಿನೀಯರಿಂಗ್ ಫೋರ್ಸ್, ಲೋಕ ಸಹಾಯಕ ಸೇನಾ ಮತ್ತು ಪ್ಯಾರಾ ಮಿಲಿಟರಿ ದಳದಲ್ಲಿ ಸೇವೆ ಸಲ್ಲಿಸಿದ ವ್ಯಕ್ತಿ ಸೇರ್ಪಡೆಯಾಗುವುದಿಲ್ಲ.

ಮತ್ತು (ಬಿ) ಕೇಂದ್ರ ಸಶಸ್ತ್ರ ದಳಗಳಲ್ಲಿ ಸೇವೆ ಸಲ್ಲಿಸುವಾಗ ಕೊಲ್ಲಲ್ಪಟ್ಟ ಅಥವಾ ಶಾಶ್ವತವಾಗಿ ದೈಹಿಕ ವಿಕಲತೆ ಹೊಂದಿದ ವ್ಯಕ್ತಿಗಳ ಕುಟುಂಬದವರು (ಸಂದರ್ಭಾನುಸಾರ ಹೆಂಡತಿ ಅಥವಾ ಗಂಡ ಮತ್ತು ಮಕ್ಕಳು ಮತ್ತು ಮಲ ಮಕ್ಕಳು) ಮಾಜಿ ಸೈನಿಕ ಮೀಸಲಾತಿಗೆ ಅರ್ಹರಾಗಿರುತ್ತಾರೆ. ಆದರೆ ಅಂತಹವರುಗಳಿಗೆ ವಯೋಮಿತಿ ಸಡಲಿಕೆಯನ್ನು ನೀಡಲಾಗುವುದಿಲ್ಲ.

ಆ) ಅಂತಹ ಸೇನೆಯಿಂದ ನಿವೃತ್ತಿ ಹೊಂದಿದ ನಂತರ ನಿವೃತ್ತಿ ವೇತನ ಪಡೆಯುತ್ತಿರುವ ಅಥವಾ

ಇ) ಸೈನಿಕ ಸೇವೆಯಿಂದ ಉಂಟಾದ ವೈದ್ಯಕೀಯ ಕಾರಣಗಳು ಅಥವಾ ಆತನ ನಿಯಂತ್ರಣ ಮೀರಿದ ಪರಿಸ್ಥಿತಿಗಳ ಮೇಲೆ ಅಂಥ ಸೇವೆಯಿಂದ ಬಿಡುಗಡೆ ಮಾಡಿರುವ ಮತ್ತು ವೈದ್ಯಕೀಯ ಅಥವಾ ಇತರ ಅಸಮರ್ಥತಾ ನಿವೃತ್ತಿ ವೇತನವನ್ನು ನೀಡಲಾಗಿರುವ ವ್ಯಕ್ತಿಯನ್ನು ಅಥವಾ

ಈ) ಆತನ ವೈಯಕ್ತಿಕ ಕೋರಿಕೆಯ ಮೇಲಲ್ಲದೆ ಸಿಬ್ಬಂದಿ ಸಂಖ್ಯೆ ಕಡಿತದ ಪ್ರತಿಫಲವಾಗಿ ಅಂಥ ಸೇವೆಯಿಂದ ಆತನನ್ನು ಬಿಡುಗಡೆಗೊಳಿಸಿರುವ ವ್ಯಕ್ತಿಯನ್ನು ಅಥವಾ

ಉ) ಆತನ ವೈಯಕ್ತಿಕ ಕೋರಿಕೆ ಮೇಲಲ್ಲದೆ ಅಥವಾ ದುರ್ವರ್ತನೆ ಅಥವಾ ಅದಕ್ಷತೆಯ ಕಾರಣದಿಂದಾಗಿ ವಜಾಗೊಳಿಸುವ ಅಥವಾ ತೆಗೆದುಹಾಕುವ ಮೂಲಕವಲ್ಲದೆ, ಅನ್ಯತಾ ನಿಯೋಜಿಸಲಾದ ನಿರ್ಧಿಷ್ಟ ಅವಧಿ ಮುಕ್ತಾಯವಾದ ತರುವಾಯ ಅಂಥ ಸೇವೆಯಿಂದ ಬಿಡುಗಡೆಗೊಳಿಸಿರುವ ಮತ್ತು ಉಪದಾನ ನೀಡಿರುವ ವ್ಯಕ್ತಿಯನ್ನು ಮತ್ತು ಗ್ರಾಚುಟಿ ಪಡೆಯುತ್ತಿರುವ ವ್ಯಕ್ತಿ ಮತ್ತು ಪ್ರಾದೇಶಿಕ ಸೇನೆಯ ಮುಂದಿನ ಪ್ರವರ್ಗಗಳ ಸಿಬ್ಬಂದಿ ಎಂದರೆ.

1. ನಿರಂತರ ಸಂಚಿತೆ ಸೇವೆ ಸಂಬಂಧಿಸಿದ ನಿವೃತ್ತಿ ವೇತನದಾರ
2. ಸೈನಿಕ ಸೇವೆಯ ಕಾರಣದಿಂದ ಅಂಗವಿಕಲರಾದ ವ್ಯಕ್ತಿಗಳನ್ನು ಮತ್ತು
3. ಶೌರ್ಯ ಪ್ರಶಸ್ತಿ ವಿಜೇತರು –ಒಳಗೊಳುತ್ತದೆ.

**ಜಿ) ಸರ್ಕಾರಿ ನೌಕರ :**

ಅಭ್ಯರ್ಥಿಯು ಕರ್ನಾಟಕ ರಾಜ್ಯ ಸರ್ಕಾರದ ಅಥವಾ ಸ್ಥಳೀಯ ಪ್ರಾಧಿಕಾರದಲ್ಲಿ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಯಾದ ಅಥವಾ ರಾಜ್ಯ ಅಧಿನಿಯಮದ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಗೊಂಡು ಕರ್ನಾಟಕ ರಾಜ್ಯ ಸರ್ಕಾರದ ಸ್ವಾಮ್ಯ ಅಥವಾ ನಿಯಂತ್ರಣದಲ್ಲಿರುವ ನಿಗಮದಲ್ಲಿ ಹುದ್ದೆ ಹೊಂದಿರುವ ಅಥವಾ ಹಿಂದೆ ಹೊಂದಿದ್ದಲ್ಲಿ ಗರಿಷ್ಟ ವಯೋಮಿತಿಯನ್ನು ಅವನು/ಅವಳು ಎಷ್ಟು ವರ್ಷಗಳ ಅವಧಿಗೆ ಆ ಹುದ್ದೆಯಲ್ಲಿ ಸೇವೆ ಸಲ್ಲಿಸುತ್ತಿರುವರೋ ಅಥವಾ ಹಿಂದೆ ಸಲ್ಲಿಸಿದ್ದರೂ ಅಷ್ಟು ವರ್ಷಗಳು ಅಥವಾ 10 ವರ್ಷಗಳ ಅವಧಿ ಅದರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳು.

**ಹೆಚ್) ಅಂಗವಿಕಲ ಅಭ್ಯರ್ಥಿಗಳು :**

ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು–1977 ರ ನಿಯಮ 9(1–ಎ) ರ ಅನ್ವಯ ರಾಜ್ಯ ಸಿವಿಲ್ ಸೇವೆಯಲ್ಲಿನ ಗ್ರೂಪ್–ಸಿ ಹುದ್ದೆಗಳ ನೇರ ನೇಮಕಾತಿಯಲ್ಲಿ ಅಂಗವಿಕಲರಿಗೆ ಶೇ. 5 ರಷ್ಟು ಸಮತಳ ಮೀಸಲಾತಿ ಕಲ್ಪಿಸಲಾಗಿದೆ. ಸರ್ಕಾರದ ಆದೇಶ ಸಂಖ್ಯೆ: ಡಿಪಿಎಆರ್.52.ಎಸ್ಆರ್ಆರ್.59, ದಿನಾಂಕ: 29/11/2002 ರಂತೆ ಮೀಸಲಾತಿ ನೀಡಲಾಗುವುದು. ಸರ್ಕಾರದ ಅಧಿಕೃತ ಜ್ಞಾಪನ ಸಂಖ್ಯೆ: ಸಿಆಸುಎ.115.ಸೆನೆನಿ.2005, ದಿನಾಂಕ: 19/11/2005 ರಲ್ಲಿ ನಿಗಧಿಪಡಿಸಿರುವ ನಮೂನೆಯಲ್ಲಿ ಅಂಗವಿಕಲತೆಯ ಬಗ್ಗೆ ಸಂಬಂಧಪಟ್ಟ ಜಿಲ್ಲಾಮಟ್ಟದ ವೈದ್ಯಕೀಯ ಮಂಡಳಿಯು ನೀಡುವ ಮೂಲ ಪ್ರಮಾಣ ಪತ್ರವನ್ನು ಹಾಗೂ ದೃಢೀಕೃತ ಪ್ರತಿಯನ್ನು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು. ಬೇರೆ ಯಾವುದೇ ನಮೂನೆಗಳಲ್ಲಿ ಪಡೆಯಲಾಗಿರುವ ಪ್ರಮಾಣ ಪತ್ರಗಳನ್ನು ಪರಿಗಣಿಸಲಾಗುವುದಿಲ್ಲ. ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್.52.ಎಸ್ಆರ್ಆರ್.99, ದಿನಾಂಕ: 29/11/2002 ಮತ್ತು ತಿದ್ದುಪಡಿ ಅಧಿಸೂಚನೆ ಸಂಖ್ಯೆ: ಡಿಪಿಎಆರ್.54.ಎಸ್ಆರ್ಆರ್.2012, ದಿನಾಂಕ: 23/06/2012 ರ ರೀತ್ಯಾ ಗ್ರಾಮಲೆಕ್ಕಿಗರ ಹುದ್ದೆಗಳಲ್ಲಿ ನಿಗಧಿತ ಪ್ರಮಾಣದ ಅಂಗವೈಕಲ್ಯವುಳ್ಳ ಅಂಗವಿಕಲರ ಮೀಸಲಾತಿಯನ್ನು ಈ ಕೆಳಕಂಡ ವರ್ಗಗಳಿಗೆ ಮಾತ್ರ ಕಲ್ಪಿಸಲಾಗಿದೆ.

1. ಕುಷ್ಟ ರೋಗದಿಂದ ಗುಣಮುಖರಾದವರು (Leprosy Cured)
2. ಶ್ರವಣ ದೋಷವುಳ್ಳವರು (Hearing impaired)
3. ದೈಹಿಕ ಅಂಗವಿಕಲರು (Locomotor disability)
4. ಮಾನಸಿಕ ಅಸ್ವಸ್ಥತೆ (Mentally ill)

ಈ ಮೇಲಿನ ಅಂಗವಿಕಲರು ಹೊರತುಪಡಿಸಿ ಇತರೆ ಅಂಗವಿಕಲತೆಯುಳ್ಳ ಅಭ್ಯರ್ಥಿಗಳು ಗ್ರಾಮಲೆಕ್ಕಿಗರ ಹುದ್ದೆಗೆ ಅರ್ಜಿ ಸಲ್ಲಿಸಲು ಅರ್ಹರಿರುವುದಿಲ್ಲ ಹಾಗೂ ಈ ವರ್ಗದ ಅಂಗವಿಕಲ ಅಭ್ಯರ್ಥಿಗಳು ಗ್ರಾಮಲೆಕ್ಕಾಧಿಕಾರಿಗಳ ಹುದ್ದೆಯಲ್ಲಿ ಕಾರ್ಯ ನಿರ್ವಹಿಸುವ ಕನಿಷ್ಠ ಸಾಮರ್ಥ್ಯ ಹೊಂದಿರಬೇಕಾಗಿರುತ್ತದೆ.

**6. ಜಾತಿ/ಮೀಸಲಾತಿ ಪ್ರಮಾಣ ಪತ್ರಗಳು:**

ಜಾತಿ ಮೀಸಲಾತಿ ಕೋರಬಯಸುವ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ ಅಭ್ಯರ್ಥಿಗಳು ನಮೂನೆ–ಡಿ ರಲ್ಲಿ, ಪ್ರವರ್ಗ–1, ಅಭ್ಯರ್ಥಿಗಳು ನಮೂನೆ–ಇ ನಲ್ಲಿ ಹಾಗೂ 2ಎ, 2ಬಿ, 3ಎ, 3ಬಿ ಅಭ್ಯರ್ಥಿಗಳು ನಮೂನೆ–ಎಫ್ ನಲ್ಲಿ ಸಂಬಂಧಿತ ತಹಶೀಲ್ದಾರ್‌ರವರಿಂದ ಪ್ರಮಾಣ ಪತ್ರವನ್ನು ಪಡೆದಿರಬೇಕು. ಈ ಪ್ರಮಾಣ ಪತ್ರವು ಈ ಹುದ್ದೆಗೆ ಅರ್ಜಿ ಸಲ್ಲಿಸಲು ನಿಗದಿಪಡಿಸಿರುವ ಕೊನೆಯ ದಿನಾಂಕದೊಳಗೆ ಪಡೆದಿರಬೇಕು/ಚಾಲ್ತಿಯಲ್ಲಿರಬೇಕು, ನಂತರ ಪಡೆದ ಪ್ರಮಾಣ ಪತ್ರಗಳನ್ನು ಪರಿಗಣಿಸುವುದಿಲ್ಲ.

**7. ಯೋಜನೆ ನಿರಾಶ್ರಿತರಾದ ಕುಟುಂಬದ ಅಭ್ಯರ್ಥಿಗಳು :**

ಯೋಜನೆಗಳಿಂದ ನಿರ್ವಸಿತರಾದ ಕುಟುಂಬದ ಅಭ್ಯರ್ಥಿಗಳಿಗೆ ಮೀಸಲಿರಿಸಿದ ಹುದ್ದೆಗಳನ್ನು ಕೋರುವ ಅಭ್ಯರ್ಥಿಗಳು ಸಂಬಂಧಿಸಿದ ತಹಶೀಲ್ದಾರ್ ರವರಿಂದ ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್.23.ಎಸ್‌ಆರ್‌ಆರ್.99, ದಿನಾಂಕ: 23/11/2000 ರನ್ವಯ ಈ ಮೀಸಲಾತಿಯಡಿಯಲ್ಲಿ ಕ್ಲೈಮು ಮಾಡುವ ಅಭ್ಯರ್ಥಿಗಳು ಸರ್ಕಾರದ ಆದೇಶದ ಸಂಖ್ಯೆ: ಸಿಆಸುಇ.44.ಸೆಸೇನಿ.2001, ದಿನಾಂಕ: 27/07/2001 ರಲ್ಲಿ ತಿಳಿಸಿರುವಂತೆ ನಿಗದಿತ ನಮೂನೆಯಲ್ಲಿ ಸಲ್ಲಿಸತಕ್ಕದ್ದು.

**8. ಮಾಜಿ ಸೈನಿಕರ ಕುಟುಂಬದ ಅಭ್ಯರ್ಥಿಗಳು :**

ಮಾಜಿ ಸೈನಿಕರು ಎನ್ನುವ ಬಗ್ಗೆ ಅಥವಾ ಭಾರತ ದೇಶದ ಒಕ್ಕೂಟದ ಸಶಸ್ತ್ರ ದಳದಲ್ಲಿ ಸೇವೆ ಸಲ್ಲಿಸುತ್ತಿರುವಾಗ ಕೊಲ್ಲಲ್ಪಟ್ಟ ಅಥವಾ ಶಾಶ್ವತವಾಗಿ ಅಂಗಹೀನರಾದ ವ್ಯಕ್ತಿಗಳ ಕುಟುಂಬದ ಸದಸ್ಯರು ಎಂಬ ಬಗ್ಗೆ ಸಕ್ಷಮ ಮಿಲಿಟರಿ ಅಧಿಕಾರಿಗಳಿಂದ/ಸಕ್ಷಮ ಪ್ರಾಧಿಕಾರದಿಂದ ಪ್ರಮಾಣ ಪತ್ರವನ್ನು ಪಡೆದಿರಬೇಕು.

**9. ಗ್ರಾಮೀಣ ಅಭ್ಯರ್ಥಿಗಳು :**

ಗ್ರಾಮೀಣ ಅಭ್ಯರ್ಥಿ ಎಂದರೆ ಒಂದು ಹುದ್ದೆಗಾಗಿ ನಿಯಮಿಸಲಾದ ಅರ್ಹತಾ ಪರೀಕ್ಷೆಯು ಎಸ್.ಎಸ್.ಎಲ್.ಸಿ., ಅಥವಾ ಉನ್ನತ ಪರೀಕ್ಷೆಯಾಗಿದ್ದಲ್ಲಿ 1ನೇ ತರಗತಿಯಿಂದ 10ನೇ ತರಗತಿವರೆಗೆ ಗ್ರಾಮಾಂತರ ಪ್ರದೇಶದಲ್ಲಿ ವ್ಯಾಸಂಗ ಮಾಡಿದ ಬಗ್ಗೆ ವ್ಯಾಸಂಗದ ಪ್ರಮಾಣ ಪತ್ರವನ್ನು ಸಂಬಂಧಪಟ್ಟ ಪ್ರಾಧಿಕಾರಿಯಿಂದ ಪಡೆದು ಲಗತ್ತಿಸತಕ್ಕದ್ದು. ಗ್ರಾಮೀಣ ಮೀಸಲಾತಿಗೆ ಒಳಪಡುವ ಪ್ರದೇಶಗಳಲ್ಲಿ ವ್ಯಾಸಂಗ ಮಾಡಿ ಉತ್ತೀರ್ಣರಾಗಿರುವವರು ಈ ಮೀಸಲಾತಿಯನ್ನು ಪಡೆಯಲು ಅರ್ಹರು. ಗ್ರಾಮೀಣ ಅಭ್ಯರ್ಥಿಗಳಿಗೆಂದು ಮೀಸಲಿರಿಸಿದ ಹುದ್ದೆಗಳನ್ನು ಕ್ಲೈಮು ಮಾಡುವ ಸಾಮಾನ್ಯ ಅರ್ಹತೆಯ ಅಭ್ಯರ್ಥಿಗಳು ನಮೂನೆ–2 ರಲ್ಲಿ ಪ್ರಮಾಣ ಪತ್ರವಲ್ಲದೆ ಮೇಲುಸ್ಥರಕ್ಕೆ ಸೇರಿಲ್ಲದಿರುವ ಬಗ್ಗೆ ನಮೂನೆ–1 ರಲ್ಲಿ ಪ್ರಮಾಣ ಪತ್ರವನ್ನು ಕಡ್ಡಾಯವಾಗಿ ಸಂಬಂಧಿತ ತಹಶೀಲ್ದಾರ್‌ರವರಿಂದ ಪಡೆದು ಅದರ ಒಂದೊಂದು ಫೋಟೋ ಪ್ರತಿಗಳನ್ನು ಇಟ್ಟುಕೊಂಡಿರಬೇಕು.

ಅಂತೆಯೇ ಗ್ರಾಮೀಣ ಮೀಸಲಾತಿ ಕೋರುವ ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ, ಪ್ರವರ್ಗ–1, ಪ್ರವರ್ಗ–2ಎ, 2ಬಿ, 3ಎ, 3ಬಿ ಮೀಸಲಾತಿಗೆ ಸೇರಿದ ಅಭ್ಯರ್ಥಿಗಳು ಕಡ್ಡಾಯವಾಗಿ ಗ್ರಾಮೀಣ ಮೀಸಲಾತಿಯ ಪ್ರಮಾಣ ಪತ್ರವು ನಮೂನೆ–2 ರಲ್ಲಿ ನಿಗದಿತ ಪ್ರಾಧಿಕಾರಿಗಳಿಂದ ಪಡೆದು ಸಂಬಂಧಪಟ್ಟ ಕ್ಷೇತ್ರ ಶಿಕ್ಷಣಾಧಿಕಾರಿಯವರಿಂದ ಮೇಲುರುಜು ಮತ್ತು ಮೊಹರು ಮಾಡಿಸಿಕೊಂಡಿರತಕ್ಕದ್ದು.

**10. ಕನ್ನಡ ಮಾಧ್ಯಮ ಅಭ್ಯರ್ಥಿಗಳು :**

ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್.71.ಎಸ್‌ಆರ್‌ಆರ್.2001, ದಿನಾಂಕ: 24/10/2002 ರಲ್ಲಿ ಹೊರಡಿಸಿದ ಕರ್ನಾಟಕ ಸರ್ಕಾರಿ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು–1977 ರ ನಿಯಮ (9)(1)(ಸಿ) ರನ್ವಯ ಅಭ್ಯರ್ಥಿಯು 1 ರಿಂದ 10ನೇ ತರಗತಿವರೆಗೆ ಕನ್ನಡ ಮಾಧ್ಯಮದಲ್ಲಿ ವ್ಯಾಸಂಗ ಮಾಡಿರುತ್ತಾರೆ ಎನ್ನುವ ಬಗ್ಗೆ ಸಂಬಂಧಪಟ್ಟ ಶಾಲೆಯ ಮುಖ್ಯೋಪಾಧ್ಯಾಯರ ಸಹಿ ಹಾಗೂ ಮೊಹರು ಪಡೆದ ಪ್ರಮಾಣ ಪತ್ರವನ್ನು ಪಡೆದುಕೊಳ್ಳತಕ್ಕದ್ದು.

**11. ಅರ್ಹತಾ ಷರತ್ತುಗಳು :**

ಅ) ಅರ್ಜಿದಾರರು ಭಾರತೀಯ ನಾಗರೀಕನಾಗಿರತಕ್ಕದ್ದು.

ಆ) ಅಭ್ಯರ್ಥಿಯು ಮಾನಸಿಕವಾಗಿ ಮತ್ತು ದೈಹಿಕವಾಗಿ ಆರೋಗ್ಯವಂತರಾಗಿರಬೇಕು ಮತ್ತು ಅವರ ನೇಮಕಾತಿಯ ಕರ್ತವ್ಯಗಳ ದಕ್ಷ ನಿರ್ವಹಣೆಗೆ ಆತಂಕವನ್ನುಂಟುಮಾಡುವ ಸಂಭವ ಇರುವ ಯಾವುದೇ ದೈಹಿಕ ನ್ಯೂನತೆಯಿಂದ ಮುಕ್ತರಾಗಿರಬೇಕು.

ಇ) ದೈಹಿಕವಾಗಿ/ಮಾನಸಿಕವಾಗಿ ಅನರ್ಹರಾಗಿದ್ದಾರೆಂಬುದಾಗಿ ವೈದ್ಯಕೀಯ ಮಂಡಳಿಯ ವರದಿಯ ಮೇಲೆ ಅಭ್ಯರ್ಥಿ ಹುದ್ದೆಗೆ ಅನರ್ಹರೆಂಬುದಾಗಿ ತಿರಸ್ಕರಿಸುವ ಪೂರ್ಣ ವಿವೇಚನೆಯನ್ನು ರಾಜ್ಯ ಸರ್ಕಾರವು ಕಾಯ್ದಿರಿಸಿಕೊಂಡಿದೆ ಮತ್ತು ಸರ್ಕಾರದ ವಿವೇಚನೆಯು ಯಾವುದೇ ವಿಧದಲ್ಲೂ ಈ ನಿಯಮಗಳ ಮೂಲಕ ಸೀಮಿತವಾಗಿರುವುದಿಲ್ಲ.

**12. ಪ್ರಮುಖವಾದ ಸೂಚನೆಗಳು :**

ಅಭ್ಯರ್ಥಿಗಳು ಕೆಳಕಂಡ ಪ್ರಮಾಣ ಪತ್ರಗಳನ್ನು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.

- ಹುದ್ದೆಗೆ ನಿಗದಿಪಡಿಸಲಾದ ವಿದ್ಯಾರ್ಹತೆಯ ಅಂಕಪಟ್ಟಿ ಪ್ರಮಾಣ ಪತ್ರ ಮತ್ತು ಕಂಪ್ಯೂಟರ್ ಜ್ಞಾನದ ಬಗ್ಗೆ ದಾಖಲೆ.
- ಜನ್ಮ ದಿನಾಂಕವನ್ನು ನಮೂದಿಸಿರುವ ಎಸ್.ಎಸ್.ಎಲ್.ಸಿ., ಅಥವಾ ತತ್ಸಮಾನ ಪರೀಕ್ಷೆಯ ಪ್ರಮಾಣ ಪತ್ರ.
- ಸೈನಿಕ ಸೇವೆಯಿಂದ ಬಿಡುಗಡೆಯಾದ/ ಮುಕ್ತಿ ಹೊಂದಿದ ಬಗೆಗಿನ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)

- ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ, ಪ್ರವರ್ಗ–1, ಪ್ರವರ್ಗ–2, 2ಬಿ, 3ಎ, 3ಬಿ ಮೀಸಲಾತಿಯ ಪ್ರಮಾಣ ಪತ್ರಗಳು (ಮೀಸಲಾತಿ ಕೋರಿದ್ದಲ್ಲಿ)
- ಗ್ರಾಮೀಣ ಮೀಸಲಾತಿ ಪ್ರಮಾಣ ಪತ್ರ ನಮೂನೆ–1 ಮತ್ತು 2 ರಲ್ಲಿ (ಮೀಸಲಾತಿ ಕೋರಿದ್ದಲ್ಲಿ)
- ಕನ್ನಡ ಮಾಧ್ಯಮದಲ್ಲಿ ವ್ಯಾಸಂಗ ಮಾಡಿದ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)
- ಯೋಜನೆಗಳಿಂದ ನಿರಾಶ್ರಿತರಾದ ಬಗ್ಗೆ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)
- ವಿಧವೆಯಾಗಿದ್ದಲ್ಲಿ ಸಕ್ಷಮ ಪ್ರಾಧಿಕಾರದಿಂದ ಪಡೆದ ಪ್ರಮಾಣ ಪತ್ರ
- ಅಂಗವಿಕಲ ಮೀಸಲಾತಿ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)

13. **ದುರ್ನಡತೆ :**

ಒಬ್ಬ ಅಭ್ಯರ್ಥಿಯು ನಕಲಿ ವ್ಯಕ್ತಿಯಾಗಿರುವನೆಂದು ಅಥವಾ ಖೋಟಾ ದಸ್ತಾವೇಜು ಅಥವಾ ತಿದ್ದಲಾದ ದಸ್ತಾವೇಜುಗಳನ್ನು ಸಲ್ಲಿಸಿರುವನೆಂದು ಅಥವಾ ತಪ್ಪು ಅಥವಾ ಸುಳ್ಳು ಹೇಳಿಕೆ ನೀಡಿರುವನೆಂದು ಅಥವಾ ವಾಸ್ತವಿಕ ಮಾಹಿತಿಯನ್ನು ಮರೆಮಾಚಿರುವನೆಂದು ಅಥವಾ ಅವರ ನೇಮಕಾತಿಯ ಸಂಬಂಧದಲ್ಲಿ ಯಾವುದೇ ಇತರ ಅಕ್ರಮ ಮತ್ತು ಅನುಚಿತ ಮಾರ್ಗವನ್ನು ಅನುಸರಿಸಿರುವುದು ಕಂಡು ಬಂದಲ್ಲಿ ಅವನು/ಅವಳು ಸ್ವತಃ ಕ್ರಿಮಿನಲ್ ವ್ಯವಹರಣೆಗಳಿಗೆ ಮತ್ತು ಶಿಸ್ತು ಕ್ರಮಕ್ಕೆ ಒಳಪಡುವುದಲ್ಲದೆ, ಹುದ್ದೆಯ ಆಯ್ಕೆಯಿಂದ ಅಭ್ಯರ್ಥಿತ್ವವನ್ನು ರದ್ದುಪಡಿಸಲಾಗುವುದು.

14. **ಇತರೆ ಸೂಚನೆಗಳು :**

1. ಅಭ್ಯರ್ಥಿಗಳಿಗೆ ಕನ್ನಡ ಭಾಷಾ ಜ್ಞಾನದ ಅರಿವು ಅವಶ್ಯಕತೆ ಕಡ್ಡಾಯವಾಗಿರುತ್ತದೆ.
2. ನೇಮಕಾತಿ ಪ್ರಕ್ರಿಯೆ ಪೂರ್ಣಗೊಳ್ಳುವ ಮುನ್ನ ಯಾವುದೇ ಸಂದರ್ಭದಲ್ಲಿ ಹುದ್ದೆಗಳ ಸಂಖ್ಯೆಯನ್ನು ಹೆಚ್ಚು ಮಾಡುವ/ಕಡಿತಗೊಳಿಸುವ ಅಥವಾ ನಿಯಮಾನುಸಾರ ಅಗತ್ಯವಾದ ಯಾವುದೇ ಹೆಚ್ಚುವರಿ ಷರತ್ತುಗಳನ್ನು ವಿಧಿಸುವ ಅಥವಾ ಸಡಿಲಗೊಳಿಸುವ ಅಧಿಕಾರ ಹಾಗೂ ಯಾವುದೇ ಕಾರಣ ನೀಡದೆ ನೇಮಕಾತಿ ಪ್ರಕ್ರಿಯೆಯನ್ನು ರದ್ದುಪಡಿಸುವ ಅಧಿಕಾರ ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ ರವರು ಕಾಯ್ದಿರಿಸಿಕೊಂಡಿರುತ್ತಾರೆ.
3. ಸರ್ಕಾರಿ ಇಲಾಖೆಯಲ್ಲಿ ಸೇವೆ ಸಲ್ಲಿಸುತ್ತಿರುವ ಅಭ್ಯರ್ಥಿಗಳು ಅರ್ಜಿಯನ್ನು ಇಲಾಖಾ ಮುಖ್ಯಸ್ಥರ ಅನುಮತಿ ಪಡೆದು ಸಲ್ಲಿಸುವುದು.
4. ಮೀಸಲಾತಿಯಡಿಯಲ್ಲಿ ಆಯ್ಕೆಯಾದ ಅಭ್ಯರ್ಥಿಗಳು ಜಾತಿ ಪ್ರಮಾಣ ಪತ್ರದ ಬಗ್ಗೆ ಜಿಲ್ಲಾಧಿಕಾರಿಗಳು (ಅಧ್ಯಕ್ಷರು, ಜಾತಿ ಮತ್ತು ಆದಾಯ ಪರಿಶೀಲನಾ ಸಮಿತಿ) ರವರಿಂದ ಸಿಂಧುತ್ವ ಪ್ರಮಾಣ ಪತ್ರ ಪಡೆದ ನಂತರ ನೇಮಕಾತಿ ಆದೇಶ ನೀಡಲಾಗುವುದು.
5. ನೇಮಕಾತಿ ಬಗ್ಗೆ ಅಂತಿಮ ತೀರ್ಮಾನವನ್ನು ನೇಮಕಾತಿ ಪ್ರಾಧಿಕಾರಿಯಾದ ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ರವರು ಕಾಯ್ದಿರಿಸಿಕೊಂಡಿರುತ್ತಾರೆ.
6. ಕಾಲೇಜಿನ ಪ್ರಾಂಶುಪಾಲರಿಂದ ಪಡೆದ ಒಂದು ನಡತೆ ಪ್ರಮಾಣ ಪತ್ರ ಹಾಗೂ ಸ್ಥಳೀಯ ಇಬ್ಬರು ಗಣ್ಯ ವ್ಯಕ್ತಿಗಳಿಂದ ಪಡೆದ 6 ತಿಂಗಳೊಳಗಿನ ಇತ್ತಿಚಿನ ನಡತೆ ಪ್ರಮಾಣ ಪತ್ರ ಲಗತ್ತಿಸಬೇಕು.
7. ಅಭ್ಯರ್ಥಿಗಳು ಆನ್‌ಲೈನ್‌ನಲ್ಲಿ ಪಡೆದ Acknowledgement ಹಾಗೂ Challan ನ್ನು ಬ್ಯಾಂಕ್‌ನಲ್ಲಿ ಪಾವತಿಸಿದ ನಂತರ ಅಭ್ಯರ್ಥಿಯ ಪ್ರತಿಯನ್ನು ಮಡಚುವುದಾಗಲೀ, ಹರಿಯುವುದಾಗಲೀ ಮಾಡದೇ ಹಾಳಾಗದಂತೆ ಎಚ್ಚರವಹಿಸತಕ್ಕದ್ದು.
8. ಸೇವೆಯಲ್ಲಿರುವ ಅಭ್ಯರ್ಥಿಗಳು ಅವರ ನೇಮಕಾತಿ ಪ್ರಾಧಿಕಾರದಿಂದ ನಿರಾಕ್ಷೇಪಣಾ ಪತ್ರವನ್ನು (No Objection Certificate) ಪಡೆದು ಮೂಲ ದಾಖಲಾತಿಗಳ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.
9. ನೇಮಕಾತಿ ಬಗ್ಗೆ ಅಂತಿಮ ತೀರ್ಮಾನವನ್ನು ನೇಮಕಾತಿ ಪ್ರಾಧಿಕಾರದ ಅಧ್ಯಕ್ಷರಾದ ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ, ಚಿಕ್ಕಬಳ್ಳಾಪುರ ಇವರು ಕಾಯ್ದಿರಿಸಿಕೊಂಡಿರುತ್ತಾರೆ.
10. ಕರ್ನಾಟಕ ಜನರಲ್ ಸರ್ವೀಸ್ (Revenue Sub-ordinated) (Cadre & Recruitment) (ತಿದ್ದುಪಡಿ) ನಿಯಮಗಳು–2008 ಮತ್ತು ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು–1977 ರ ಪ್ರಕಾರ ಅಭ್ಯರ್ಥಿಯನ್ನು ಅವರು ಪಿ.ಯು.ಸಿ. ಅಥವಾ ಸಿಬಿಎಸ್‌ಸಿ. ಅಥವಾ ಐಸಿಎಸ್‌ಇ ನಡೆಸುವ 12ನೇ ತರಗತಿ ಪರೀಕ್ಷೆಯಲ್ಲಿ ಪಡೆದ ಅಂಕಗಳ (on merit) ಮತ್ತು ಮೀಸಲಾತಿ ಆಧಾರದ ಮೇಲೆ ಮಾತ್ರ ಆಯ್ಕೆ ಮಾಡಲಾಗುವುದು. ಮುಕ್ತ ವಿದ್ಯಾಲಯದಿಂದ ನೀಡಲಾದ ಪ್ರಮಾಣ ಪತ್ರಗಳನ್ನು ಹಾಗೂ ಗಳಿಸಿದ ಅಂಕಗಳನ್ನು ಪರಿಗಣಿಸಲಾಗುವುದಿಲ್ಲ.
11. ನೇಮಕಾತಿಯು ಸಂಪೂರ್ಣವಾಗಿ ಮೆರಿಟ್ ಮತ್ತು ಮೀಸಲಾತಿ ನಿಯಮಗಳನ್ವಯ ಮಾತ್ರವೇ ನಡೆಯುತ್ತದೆ.
12. 1:5 ಅನುಪಾತದಲ್ಲಿ Provisional ಪಟ್ಟಿ ಪ್ರಕಟಿಸಲಾಗುವುದು ಹಾಗೂ ಅಭ್ಯರ್ಥಿಯ ಹೆಸರು Provisional List ನಲ್ಲಿ ನಮೂದಿಸಿದ ಮಾತ್ರಕ್ಕೆ ಅವರ ಆಯ್ಕೆ ಅಂತಿಮವಾಗಿದೆ ಎಂದು ಭಾವಿಸತಕ್ಕದ್ದಲ್ಲ. ಆಯ್ಕೆಯ ಸಂಬಂಧವಾಗಿ ಈ ಕಛೇರಿಯೊಂದಿಗೆ ಯಾವುದೇ ಪತ್ರ ವ್ಯವಹಾರ ನಡೆಸಲು ಅವಕಾಶ ಇರುವುದಿಲ್ಲ.
13. ಅಂತಿಮವಾಗಿ ಅಭ್ಯರ್ಥಿಗಳಿಗೆ ನೇಮಕಾತಿ ಆದೇಶಗಳನ್ನು ನೀಡುವ ಮುನ್ನ ಯಾವುದೇ ಹಂತದಲ್ಲಿ ಯಾವುದೇ ಕಾರಣ/ಮಾಹಿತಿ ನೀಡದೆ ಈ ನೇಮಕಾತಿ ಪ್ರಕ್ರಿಯೆಯನ್ನು ಮುಂದೂಡುವ ಅಥವಾ ರದ್ದುಪಡಿಸುವ ಅಥವಾ ವಿಧಿಸಲಾಗಿರುವ ಯಾವುದೇ ಷರತ್ತನ್ನು ಸಡಿಲಗೊಳಿಸುವ ಅಥವಾ ಹೆಚ್ಚುವರಿ ಷರತ್ತನ್ನು ವಿಧಿಸುವ, ತುಂಬಲಾಗುವ ಹುದ್ದೆಗಳ ಸಂಖ್ಯೆಯನ್ನು ಬದಲಾಯಿಸುವ/ನಿರ್ಣಯಿಸುವ ಅಧಿಕಾರವನ್ನು ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ ರವರು ಕಾಯ್ದಿರಿಸಿಕೊಂಡಿರುತ್ತಾರೆ.

**ಡಾ॥ ವಿಶಾಲ್ ಆರ್. ಭಾ.ಆ.ಸೇ.,**

**ಅಧ್ಯಕ್ಷರು**

ಗ್ರಾಮಲೆಕ್ಕಿಗರ ನೇಮಕಾತಿ ಮತ್ತು ಆಯ್ಕೆ ಪ್ರಾಧಿಕಾರ

ಹಾಗೂ ಜಿಲ್ಲಾಧಿಕಾರಿಗಳು, ಚಿಕ್ಕಬಳ್ಳಾಪುರ ಜಿಲ್ಲೆ.

**PR.78**

**S.C.50**

ಸರ್ಕಾರಿ ಕೇಂದ್ರ ಮುದ್ರಣಾಲಯ, ಘಟಕ–2, ಬೆಂಗಳೂರು